RNI No. **KARBIL/2001/47147**

# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

| ಸಂಪುಟ ೧೪೮<br>Volume 148 | ಬೆಂಗಳೂರು, ಗುರುವಾರ, ಸೆಪ್ಟೆಂಬರ್ ೫, ೨೦೧೩ (ಭಾದ್ರಪದ ೧೪, ಶಕ ವರ್ಷ ೧೯೩೫)<br>Bangalore, Thursday, September 5, 2013 ( Bhadrapada 14, Shaka Varsha 1935) | ಸಂಚಿಕೆ ೩೬<br>Issue 36 |
|---|---|---|

## ಭಾಗ ೫

## ಸರ್ಕಾರದ ಮತ್ತು ಖಾಸಗಿ ಜಾಹೀರಾತುಗಳು, ಲೋಕಸೇವಾ ಆಯೋಗದ ಜಾಹೀರಾತುಗಳು, ನೇಮಕಾತಿ ಸಮಿತಿಗಳ ಜಾಹೀರಾತುಗಳು

### ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರವರ ಕಛೇರಿ, ಚಾಮರಾಜನಗರ

**ಅಧಿಸೂಚನೆ ಸಂಖ್ಯೆ. ಎಡಿಎಮ್ಎನ್ / 1875 /2013 ದಿನಾಂಕ: 02.08.2013**

**ವಿಷಯ:** ಚಾಮರಾಜನಗರ ಜಿಲ್ಲಾ ನ್ಯಾಯಾಂಗ ಘಟಕದಲ್ಲಿ ಖಾಲಿ ಇರುವ ಶೀಘ್ರಲಿಪಿಗಾರರ 5 ಬ್ಯಾಕ್‌ಲಾಗ್ ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ಭರ್ತಿ ಮಾಡುವ ಬಗ್ಗೆ.

**ಉಲ್ಲೇಖ:**
1. ಗೌರವಾನ್ವಿತ ಕರ್ನಾಟಕ ಉಚ್ಚ ನ್ಯಾಯಾಲಯದ ಅನುಮತಿ ಪತ್ರ ಸಂಖ್ಯೆ:LCA–II 128/2012, ದಿನಾಂಕ 26–07–2013.
2. ಗೌರವಾನ್ವಿತ ಕರ್ನಾಟಕ ಉಚ್ಚ ನ್ಯಾಯಾಲಯದ ಅನುಮತಿಯ ಮೇರೆಗೆ ಹೊರಡಿಸಲಾದ ಈ ಕಛೇರಿ ಅಧಿಸೂಚನೆ ಸಂಖ್ಯೆ:ಎಡಿಎಮ್ಎನ್/877/2013, ದಿನಾಂಕ 30–03–2013 ರಲ್ಲಿ ಭರ್ತಿಯಾಗದೆ ಉಳಿದಿರುವ 5 ಶೀಘ್ರಲಿಪಿಗಾರರ ಬ್ಯಾಕ್‌ಲಾಗ್ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು.
3. ದಿನಾಂಕ 01–08–2013 ಕಛೇರಿ ಟಿಪ್ಪಣಿ ಮೇಲಿನ ಆದೇಶ.

ಚಾಮರಾಜನಗರ ಜಿಲ್ಲಾ ನ್ಯಾಯಾಂಗ ಘಟಕದ ಜಿಲ್ಲಾ ನ್ಯಾಯಾಲಯ ಮತ್ತು ಅಧೀನ ನ್ಯಾಯಾಲಯಗಳಲ್ಲಿ ತೆರವಾಗಿರುವ ಶೀಘ್ರಲಿಪಿಗಾರರ 5 ಬ್ಯಾಕ್‌ಲಾಗ್ ಹುದ್ದೆಗಳನ್ನು ಭರ್ತಿ ಮಾಡಲು ಅರ್ಹ ಅಭ್ಯರ್ಥಿಗಳಿಂದ ಅರ್ಜಿಗಳನ್ನು ಆಹ್ವಾನಿಸಿದೆ. ಈ ಅಧಿಸೂಚನೆ0ಯೊಡನೆ ಲಗತ್ತಿಸಿರುವ ಅರ್ಜಿ ನಮೂನೆ0ಯ ಬೆರಳಚ್ಚು ಪ್ರತಿ/ಗಣಕೀಕೃತ ಪ್ರತಿಯಲ್ಲಿ ಅಭ್ಯರ್ಥಿಗಳು ತಮ್ಮ ಸ್ವಂತ ಕೈ ಬರಹದಿಂದ ಎಲ್ಲಾ ಅಂಕಣಗಳನ್ನು ಜಾಗರೂಕತೆಯಿ0ದ ಭರ್ತಿ ಮಾಡಿ ಸಂಬಂಧಪಟ್ಟ ದಾಖಲೆಗಳ ನಕಲುಪ್ರತಿಗಳೊಡನೆ ದಿನಾಂಕ 07–09–2013 ರಂದು ಸ0ಜೆ 5 ಗಂಟೆಯೊಳಗೆ ಈ ಕಛೇರಿಗೆ ಸಲ್ಲಿಸತಕ್ಕದ್ದು.

**ಅರ್ಜಿಗಳನ್ನು ಸ್ವೀಕರಿಸಲು ಕೊನೆಯ ದಿನಾಂಕ: 07. 09 .2013 ರ ಸಂಜೆ 5.00 ಗಂಟೆ**

**ಅರ್ಜಿ ಸಲ್ಲಿಸಬೇಕಾದ ವಿಳಾಸ :** ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಜಿಲ್ಲಾ ಮತ್ತು ಸತ್ರ ನ್ಯಾಯಾಲಯ, ಚಾಮರಾಜನಗರ.

**ಹುದ್ದೆಯ ಪದನಾಮ : ಶೀಘ್ರಲಿಪಿಗಾರರು**

**ಖಾಲಿ ಹುದ್ದೆಗಳ ಸಂಖ್ಯೆ :** 05 ಹಿಂಬಾಕಿ ಹುದ್ದೆಗಳು

**ವೇತನಶ್ರೇಣಿ:** 14550–350–15600–400–17200–450–19000–500–21000–600–24600–700–26700 ಹಾಗೂ ಲಭ್ಯವಿರುವ ಇತರೆ ಭತ್ಯೆಗಳು.

| ವರ್ಗೀಕರಣ | ಇತರೆ | ಮಹಿಳೆ | ಗ್ರಾಮೀಣ | ಅಂಗವಿಕಲ | ಒಟ್ಟು |
|---|---|---|---|---|---|
| ಪರಿಶಿಷ್ಟ ಜಾತಿ | – | – | 1 (ಹಿಂಬಾಕಿ ಹುದ್ದೆ) | – | 1 |
| ಪರಿಶಿಷ್ಟ ಪಂಗಡ | 1 (ಹಿಂಬಾಕಿ ಹುದ್ದೆ ) | – | – | – | 1 |
| ಪ್ರವರ್ಗ – II (ಎ) | – | 1( ಹಿಂಬಾಕಿ ಹುದ್ದೆ ) | – | – | 1 |
| ಪ್ರವರ್ಗ – II (ಬಿ) | 1 ( ಹಿಂಬಾಕಿ ಹುದ್ದೆ ) | – | – | – | 1 |
| ಸಾಮಾನ್ಯ ವರ್ಗ | – | – | – | 1 * (ಹಿಂಬಾಕಿ ಹುದ್ದೆ ) | 1 |
| **ಒಟ್ಟು** | **2** | **1** | **1** | **1** | **5** |

* ಚಲನವಲನ ವೈಕಲ್ಯವುಳ್ಳ ಅಂಗವಿಕಲ ಅಭ್ಯರ್ಥಿಗಳು

**ಶೈಕ್ಷಣಿಕ ವಿದ್ಯಾರ್ಹತೆ:**

1. ಎಸ್‌ಎಸ್‌ಎಲ್‌ಸಿ ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರತಕ್ಕದ್ದು. ಕರ್ನಾಟಕ ಪ್ರೌಢಶಿಕ್ಷಣ ಪರೀಕ್ಷಾ ಮಂಡಳಿ ವತಿಯಿಂದ ನಡೆಸುವ ಹಿರಿಯ ದರ್ಜೆ ( **Senior Grade)** ಕನ್ನಡ ಮತ್ತು ಆಂಗ್ಲ ಭಾಷೆಗಳ ಬೆರಳಚ್ಚು ವಿಷಯಗಳಲ್ಲಿ ತೇರ್ಗಡೆ ಹೊಂದಿರಬೇಕು ಅಥವಾ ತತ್ಸಮಾನ ವಿದ್ಯಾರ್ಹತೆ.

2. ಕರ್ನಾಟಕ ಪ್ರೌಢಶಿಕ್ಷಣ ಪರೀಕ್ಷಾ ಮಂಡಳಿ ವತಿಯಿಂದ ನಡೆಸುವ ಹಿರಿಯ ದರ್ಜೆ (Senior Grade) ಕನ್ನಡ ಮತ್ತು ಆಂಗ್ಲ ಭಾಷೆಗಳ ಶೀಘ್ರಲಿಪಿ (**Short Hand**) ವಿಷಯಗಳಲ್ಲಿ ತೇರ್ಗಡೆ ಹೊಂದಿರಬೇಕು ಅಥವಾ ತತ್ಸಮಾನ ವಿದ್ಯಾರ್ಹತೆ.

**ಆಯ್ಕೆ ವಿಧಾನ :** ನಿಗದಿತ ಶೈಕ್ಷಣಿಕ ಅರ್ಹತಾ ಪರೀಕ್ಷೆಗಳಲ್ಲಿ ಗಳಿಸಿರುವ ಒಟ್ಟು ಶೇಕಡಾವಾರು ಅಂಕಗಳು ಮತ್ತು ನಿಮಿಷ ಒಂದಕ್ಕೆ 120 ಪದಗಳ ದರದಲ್ಲಿ 5 ನಿಮಿಷಗಳ ಉಕ್ತಲೇಖನವನ್ನು ತೆಗೆದುಕೊಂಡು, ಉಕ್ತಲೇಖನವನ್ನು 45 ನಿಮಿಷಗಳಲ್ಲಿ ಅನುಲಿಪಿ ಮಾಡುವ ಅರ್ಹತಾ ಪರೀಕ್ಷೆಯಲ್ಲಿ ಗಳಿಸುವ ಅಂಕಗಳು ಮತ್ತು ಸಂದರ್ಶನದಲ್ಲಿ ಗಳಿಸುವ ಅಂಕಗಳ ಆಧಾರದ ಮೇಲೆ ಆಯ್ಕೆ ಮಾಡಲಾಗುವುದು.

**ಟಿಪ್ಪಣಿ:** ಅರ್ಹತಾ ಪರೀಕ್ಷೆಯು ಗರಿಷ್ಠ 100 ಅಂಕಗಳನ್ನು ಒಳಗೊಂಡಿದ್ದು, ಅದರಲ್ಲಿ ತೇರ್ಗಡೆಯಾಗಲು ಕನಿಷ್ಠ 50 ಅಂಕಗಳನ್ನು ಪಡೆಯಬೇಕು ಮತ್ತು ಸಂದರ್ಶನವು 05 ಅಂಕಗಳನ್ನೊಳಗೊಂಡಿರುತ್ತದೆ.

ಮೇಲ್ಕಂಡ ಹುದ್ದೆಗಳನ್ನು ಕರ್ನಾಟಕ ಅಧೀನ ನ್ಯಾಯಾಲಯಗಳ (ಲಿಪಿಕ ಮತ್ತು ಇತರೆ ಹುದ್ದೆಗಳ) ನೇಮಕಾತಿ ನಿಯಮಗಳು 1982 ಮತ್ತು ಕರ್ನಾಟಕ ಅಧೀನ ನ್ಯಾಯಾಲಯಗಳ (ಲಿಪಿಕ ಮತ್ತು ಇತರೆ ಹುದ್ದೆಗಳು) ನೇಮಕಾತಿ (ತಿದ್ದುಪಡಿ) ನಿಯಮಗಳು 2007ರ ಅನ್ವಯ ನೇರ ನೇಮಕಾತಿಯ ಮೂಲಕ ಆಯ್ಕೆ ಮಾಡಲಾಗುವುದು ಹಾಗೂ ಕಾಲಕಾಲಕ್ಕೆ ಚಾಲ್ತಿಯಲ್ಲಿರುವ ನಿಯಮಾನುಸಾರ ಆಯ್ಕೆ ಮಾಡಲಾಗುವುದು.

**ಪರಿವೀಕ್ಷಣಾ ಅವಧಿ :** ಆಯ್ಕೆಯಾದ ಅಭ್ಯರ್ಥಿಗಳನ್ನು ನೇಮಕಾತಿ ನಿಯಮಗಳಂತೆ 2 ವರ್ಷಗಳ ಕಾಲ ಪರಿವೀಕ್ಷಣಾ ಅವಧಿಯಲ್ಲಿಡಲಾಗುವುದು. ಈ ಅವಧಿಯಲ್ಲಿ ಶೀಘ್ರಲಿಪಿಗಾರರ ಹುದ್ದೆಗೆ ನಿಗದಿಪಡಿಸಿರುವ ಇಲಾಖಾ ಪರೀಕ್ಷೆಗಳಲ್ಲಿ ಮತ್ತು ಕನ್ನಡ ಭಾಷಾ ಪರೀಕ್ಷೆಯಲ್ಲಿ ಉತ್ತೀರ್ಣರಾಗಬೇಕು.

**ವಯೋಮಿತಿ :**

1. ಅರ್ಜಿಗಳನ್ನು ಸ್ವೀಕರಿಸಲು ನಿಗದಿಪಡಿಸಿದ ಕೊನೆಯ ದಿನಾಂಕದಂದು ಅಭ್ಯರ್ಥಿಯು ಕನಿಷ್ಠ 18 ವರ್ಷ ವಯಸ್ಸನ್ನು ಪೂರೈಸಿರತಕ್ಕದ್ದು ಮತ್ತು ಈ ಕೆಳಕಂಡಂತೆ ಗರಿಷ್ಠ ವಯಸ್ಸನ್ನು ಮೀರಿರಕೂಡದು.

**ಗರಿಷ್ಠ ವಯೋಮಿತಿ :**

| | |
|---|---|
| ಸಾಮಾನ್ಯ ವರ್ಗ | 35 ವರ್ಷ ಮೀರಿರಬಾರದು |
| ಪ್ರವರ್ಗ 2ಎ, 2ಬಿ, 3ಎ, 3ಬಿ | 38 ವರ್ಷ ಮೀರಿರಬಾರದು |
| ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ / ಪ್ರವರ್ಗ – 1 | 40 ವರ್ಷ ಮೀರಿರಬಾರದು |

2. ಸರ್ಕಾರಿ ಸೇವೆಯಲ್ಲಿರುವವರಿಗೆ, ವಿಧವೆಯರಿಗೆ, ಮಾಜಿ ಸೈನಿಕರಿಗೆ, ಅಂಗವಿಕಲರಿಗೆ ಹಾಗೂ ಜೀತ ಕಾರ್ಮಿಕರಿಗೆ ನಿಯಮಾನುಸಾರ ವಯೋಮಿತಿಯಲ್ಲಿ ಸಡಿಲಿಕೆ ನೀಡಲಾಗುವುದು (ಈ ಬಗ್ಗೆ ಮೀಸಲಾತಿ ಕೋರಿದ್ದಲ್ಲಿ ನಿಗದಿ ಪಡಿಸಿದ ಪ್ರಮಾಣಪತ್ರ ಸಲ್ಲಿಸಬೇಕು
3. ಜನ್ಮ ದಿನಾಂಕವನ್ನು ನಮೂದಿಸಿರುವ ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯ ಪ್ರಮಾಣ ಪತ್ರ / ವರ್ಗಾವಣೆ ಪ್ರಮಾಣ ಪತ್ರ / ಜನನ ದಿನಾಂಕವನ್ನು ತೋರಿಸುವ ಸಂಚಿತ ದಾಖಲೆಯ ಉಧೃತ ಭಾಗದ ಪ್ರತಿ ಸಲ್ಲಿಸಬೇಕು.
4. ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ, ಪ್ರವರ್ಗ – 1, 2ಎ, 2ಬಿ, 3ಎ, 3ಬಿ, ಗಳ ಮೀಸಲಾತಿ ಪ್ರಮಾಣಪತ್ರಗಳನ್ನು ಪ್ರಸ್ತುತ ಚಾಲ್ತಿಯಲ್ಲಿರುವ ನಮೂನೆಗಳಲ್ಲಿ ಸಲ್ಲಿಸಬೇಕು. (ಮೀಸಲಾತಿ ಕೋರಿದ್ದಲ್ಲಿ)
5. ಶಾಲಾ / ಕಾಲೇಜಿನ ಮುಖ್ಯೋಪಾಧ್ಯಾಯರು/ಪ್ರಾಂಶುಪಾಲರಿಂದ ಪಡೆದ ಒಂದು ನಡತೆ ಪ್ರಮಾಣ ಪತ್ರ ಹಾಗೂ ತಮ್ಮ ಸಂಬಂಧಿಕರಲ್ಲದ ಇಬ್ಬರು ಸ್ಥಳೀಯ ಗಣ್ಯ ವ್ಯಕ್ತಿಗಳಿಂದ ಪಡೆದ 6 ತಿಂಗಳ ಇತ್ತೀಚಿನ ಎರಡು ನಡತೆ ಪ್ರಮಾಣ ಪತ್ರಗಳ ಪ್ರತಿ ಸಲ್ಲಿಸಬೇಕು. (ಗಣ್ಯ ವ್ಯಕ್ತಿಗಳ ರುಜುವಿನಡಿಯಲ್ಲಿ ದಿನಾಂಕ ದೊಡನೆ ಹೆಸರು ಮತ್ತು ಮೊಹರು ಕಡ್ಡಾಯವಾಗಿ ಇರತಕ್ಕದ್ದು)
6. ಅಂಗವಿಕಲ ಮೀಸಲಾತಿಯನ್ನು ಕೋರುವ ಅಭ್ಯರ್ಥಿಗಳು ವೈದ್ಯಕೀಯ ಪ್ರಮಾಣ ಪತ್ರವನ್ನು ದಿನಾಂಕ 19.11.2005ರ ಸರ್ಕಾರದ ಅಧಿಕೃತ ಜ್ಞಾಪನಾ ಸಂಖ್ಯೆ:ಸಿಆಸುಇ/115/ಸೇನೆನಿ/ 2005 ರಲ್ಲಿ ನಿಗದಿಪಡಿಸಿದ ನಮೂನೆಯಲ್ಲಿ ಅಂಗವಿಕಲತೆಯ ಬಗ್ಗೆ ಜಿಲ್ಲಾ ಮಟ್ಟದ ವೈದ್ಯಕೀಯ ಮಂಡಳಿಯಿಂದ ಪಡೆದ ಪ್ರಮಾಣ ಪತ್ರದ ಪ್ರತಿಯನ್ನು ಸಲ್ಲಿಸಬೇಕು.
7. ಗ್ರಾಮೀಣ ಮೀಸಲಾತಿಯನ್ನು ಕೋರುವ ಅಭ್ಯರ್ಥಿಗಳು ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ/96/ ಸೇನನಿ /2005, ದಿನಾಂಕ: 10.08.2005ರ ಪ್ರಕಾರ ನಿಗದಿತ ನಮೂನೆ–2ರಲ್ಲಿ ಅಧಿಕೃತ ಅಧಿಕಾರಿಗಳಿಂದ ಪಡೆದು ಅದನ್ನು ಸಂಬಂಧಿಸಿದ ಕ್ಷೇತ್ರ ಶಿಕ್ಷಣಾಧಿಕಾರಿಗಳಿಂದ ಮೇಲು ಸಹಿ ಮಾಡಿಸಿ ಸಲ್ಲಿಸಬೇಕು. ಗ್ರಾಮೀಣ ಮೀಸಲಾತಿ ಕೋರುವ ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ ಹಾಗೂ ಹಿಂದುಳಿದ ವರ್ಗಗಳಿಗೆ ಸೇರಿದ ಅಭ್ಯರ್ಥಿಗಳ ಮೀಸಲಾತಿ ಪ್ರಮಾಣ ಪತ್ರಗಳು ತಿರಸ್ಕೃತಗೊಂಡಲ್ಲಿ ಅವರು ಗ್ರಾಮೀಣ ಮೀಸಲಾತಿಗೂ ಅನರ್ಹರಾಗುತ್ತಾರೆ.
8. ಗ್ರಾಮೀಣ ಮೀಸಲಾತಿಯನ್ನು ಕೋರುವ ಸಾಮಾನ್ಯ ವರ್ಗದ ಅಭ್ಯರ್ಥಿಗಳು ಪ್ರಮಾಣ ಪತ್ರ ನಮೂನೆ–2ರ ಜೊತೆ ನಮೂನೆ –1 ರಲ್ಲೂ ಸಹ ದೃಢೀಕರಣ ಪತ್ರವನ್ನು ಸಲ್ಲಿಸುವುದು.

**ಅಭ್ಯರ್ಥಿಗಳಿಗೆ ಸೂಚನೆ :**

1. ಅಭ್ಯರ್ಥಿಯು ಈ ಅಧಿಸೂಚನೆಯಲ್ಲಿ ಲಗತ್ತಿಸಿದ ನಿಗದಿತ ಅರ್ಜಿ ನಮೂನೆಯಲ್ಲಿ ಬೆರಳಚ್ಚು ಮಾಡಿಸಿದ ಅಥವಾ ಗಣಕೀಕೃತ ಅರ್ಜಿಯನ್ನು ತನ್ನ ಕೈ ಬರವಣಿಗೆಯಲ್ಲಿ ಭರ್ತಿ ಮಾಡಿ ಸಲ್ಲಿಸತಕ್ಕದ್ದು. ಸರಿಯಾಗಿ ಅಂಕಣಗಳನ್ನು ಭರ್ತಿಮಾಡದೇ ಇರುವ ಅರ್ಜಿಗಳನ್ನು ತಿರಸ್ಕರಿಸಲಾಗುವುದು.
2. ಈ ಹುದ್ದೆಗೆ ವಿವಿಧ ಮೀಸಲಾತಿಯಡಿಗಳಲ್ಲಿ ಅರ್ಜಿ ಸಲ್ಲಿಸುವವರು ಪ್ರತ್ಯೇಕವಾಗಿ ಅರ್ಜಿಗಳನ್ನು ಸಲ್ಲಿಸುವುದು. ಆ ಅರ್ಜಿಗಳಲ್ಲಿ ಕಡ್ಡಾಯವಾಗಿ ಯಾವ ವರ್ಗ/ಮೀಸಲಾತಿಯಡಿಯಲ್ಲಿ ಅರ್ಜಿಗಳನ್ನು ಸಲ್ಲಿಸುತ್ತಿರುವಿರಿ ಎಂಬುದನ್ನು ಸ್ಪಷ್ಟವಾಗಿ ನಮೂದಿಸುವುದು.
3. ಅಭ್ಯರ್ಥಿಯು ಇತ್ತೀಚಿನ ಪಾಸ್‌ಪೋರ್ಟ್ ಸೈಜ್ ಫೋಟೋವನ್ನು ಅರ್ಜಿ ನಮೂನೆಯಲ್ಲಿ ತೋರಿಸಿರುವ ಜಾಗದಲ್ಲಿ ಅಂಟಿಸಿ ಅದರ ಮೇಲೆ ಸಹಿ ಮಾಡತಕ್ಕದ್ದು.
4. ಅರ್ಜಿ ನಮೂನೆಯೊಂದಿಗೆ ಸಲ್ಲಿಸಬೇಕಾಗಿರುವ ಶೈಕ್ಷಣಿಕ ವಿದ್ಯಾರ್ಹತೆಯ ಅಂಕಪಟ್ಟಿಗಳನ್ನು ಹಾಗೂ ಇತರೆ ಪ್ರಮಾಣ ಪತ್ರಗಳನ್ನು ಸ್ವಯಂ ದೃಢೀಕರಿಸತಕ್ಕದ್ದು. ಅರ್ಜಿಯೊಂದಿಗೆ ಮೂಲ ಪ್ರತಿಗಳನ್ನು ಲಗತ್ತಿಸುವ ಅವಶ್ಯಕತೆ ಇರುವುದಿಲ್ಲ. ಲಗತ್ತಿಸಿದ ಪ್ರಮಾಣ ಪತ್ರಗಳು ಅರ್ಜಿ ಸಲ್ಲಿಸುವ ದಿನಾಂಕದ ಒಳಗೆ ಪಡೆದಿರಬೇಕು.

5. ಅರ್ಜಿಗಳನ್ನು ಸ್ವೀಕರಿಸಲು ನಿಗದಿಪಡಿಸಿದ ಕೊನೆಯ ದಿನಾಂಕವು ಸಾರ್ವತ್ರಿಕ ರಜಾ ದಿನವಾಗಿ ಘೋಷಿಸಲ್ಪಟ್ಟರೆ ಆ ದಿನಾಂಕದ ಮಾರನೆಯ ಕೆಲಸದ ದಿನವು ಅರ್ಜಿಗಳನ್ನು ಸ್ವೀಕರಿಸಲು ಕೊನೆಯ ದಿನಾಂಕವಾಗುವುದು.

**ಇತರೆ ಸೂಚನೆಗಳು :**

1. ಅಭ್ಯರ್ಥಿಗಳು ನೇಮಕಾತಿ ಸಂಬಂಧದಲ್ಲಿ ಯಾವುದೇ ಅಕ್ರಮ ಮತ್ತು ಅನುಚಿತ ಮಾರ್ಗವನ್ನು ಅನುಸರಿಸುವುದು ಕಂಡು ಬಂದಲ್ಲಿ ಅಂತಹವರನ್ನು ನೇಮಕಾತಿಗೆ ಪರಿಗಣಿಸಲಾಗುವುದಿಲ್ಲ.
2. ಅಪೂರ್ಣವಾಗಿರುವ, ಸಹಿ ಮಾಡದ ಮತ್ತು ವಿದ್ಯಾರ್ಹತೆ, ಮೀಸ ಲಾತಿ ಹಾಗೂ ವಯೋಮಿತಿ ರಿಯಾಯಿತಿ ಬಗ್ಗೆ ಸಂಬಂಧಪಟ್ಟ ದಾಖಲೆಗಳನ್ನು ಹೊಂದಿರದ ಅರ್ಜಿಗಳನ್ನು ತಿರಸ್ಕರಿಸಲಾಗುವುದು.
3. ಸರ್ಕಾರಿ ಮತ್ತು ಅರೆ ಸರ್ಕಾರಿ ಸೇವೆಯಲ್ಲಿರುವ ಅಭ್ಯರ್ಥಿಗಳು ತಮ್ಮ ನೇಮಕಾತಿ ಪ್ರಾಧಿಕಾರದಿಂದ ನಿರಾಕ್ಷೇಪಣಾ ಪ್ರಮಾಣ ಪತ್ರವನ್ನು ಪಡೆದು, ಅರ್ಜಿಗಳನ್ನು ಸಂಬಂಧಿತ ನೇಮಕಾತಿ ಪ್ರಾಧಿಕಾರದ ಮೂಲಕ ಕಳುಹಿಸಬೇಕು.
4. ಅರ್ಜಿದಾರರು ದಪ್ಪ ಅಕ್ಷರಗಳಲ್ಲಿ ಲಕೋಟೆಯ ಮೇಲೆ ಹುದ್ದೆಯ ಹೆಸರನ್ನು ಕಡ್ಡಾಯವಾಗಿ ನಮೂದಿಸತಕ್ಕದ್ದು.
5. ಅಭ್ಯರ್ಥಿಗಳು ತಮ್ಮ ಅರ್ಜಿಯೊಂದಿಗೆ 5–00 ರೂಪಾಯಿ ಅಂಚೆ ಮುದ್ರಾಂಕ (ಪೋಸ್ಟಲ್ ಸ್ಟ್ಯಾಂಪ್) ವನ್ನು ಹೊಂದಿರುವ ಸ್ವ – ವಿಳಾಸದ ಲಕೋಟೆಯನ್ನು ಸಲ್ಲಿಸತಕ್ಕದ್ದು.
6. ಅಭ್ಯರ್ಥಿಗೆ ಸಂದರ್ಶನಕ್ಕೆ ಹಾಜರಾಗಲು ಮಾಹಿತಿ ಸಿಗದಿದ್ದ ಪಕ್ಷದಲ್ಲಿ ಅವರು ಸಂದರ್ಶನಕ್ಕೆ ಹಾಜರಾಗಲು ಅನರ್ಹರೆಂದು ತಿಳಿಯತಕ್ಕದ್ದು. ಈ ಬಗ್ಗೆ ಕಛೇರಿಯೊಂದಿಗೆ ಯಾವುದೇ ಪತ್ರ ವ್ಯವಹಾರವನ್ನು ನಡೆಸಲು ಆಸ್ಪದವಿರುವುದಿಲ್ಲ.
7. ವಿವರಗಳನ್ನು ಕಾಲಂಗಳಲ್ಲಿ ಭರ್ತಿ ಮಾಡಿ ಬರೆದು ಅರ್ಜಿಗಳನ್ನು ಅಂಚೆ ಮೂಲಕ ಸಲ್ಲಿಸುವುದು ಅಥವಾ ಖುದ್ದಾಗಿ ತಂದು ಸಲ್ಲಿಸಿದಲ್ಲಿ ಈ ಕಛೇರಿಯ ವೇಳೆಯಲ್ಲಿ ಮಾತ್ರ ಸ್ವೀಕರಿಸಲಾಗುವುದು.
8. ನೈತಿಕ ದುರ್ನಡತೆಯಿಂದಾಗಿ / ನೀತಿಬಾಹಿರ ಚಟುವಟಿಕೆಗಳಿಂದಾಗಿ ನ್ಯಾಯಾಲಯದಿಂದ ಶಿಕ್ಷೆಗೊಳಪಟ್ಟಿರುವ ವ್ಯಕ್ತಿ ಅಥವಾ ರಾಜ್ಯ / ಕೇಂದ್ರ / ಸ್ಥಳೀಯ ಸಂಸ್ಥೆ ಕಛೇರಿಗಳಲ್ಲಿ ನೈತಿಕ ದುರ್ನಡತೆಯಿಂದಾಗಿ ಅಥವಾ ನೀತಿಬಾಹಿರ ಚಟುವಟಿಕೆಗಳಲ್ಲಿ ಒಳಗಾಗಿ ಅಥವಾ ಆಯ್ಕೆಯಾದ ಅಭ್ಯರ್ಥಿಯು ಬದಲಿಯಾಗಿ ಕಾರ್ಯ ನಿರ್ವಹಿಸುತ್ತಿದ್ದ ಸಂದರ್ಭದಲ್ಲಿ ಕಾನೂನು ಬಾಹಿರ / ನೀತಿ ಬಾಹಿರ ಚಟುವಟಿಕೆಗಳಲ್ಲಿ ತೊಡಗಿ ಸೇವೆಯಿಂದ ತೆಗೆದು ಹಾಕಿದ್ದಲ್ಲಿ / ವಜಾ ಮಾಡಲ್ಪಟ್ಟಿದ್ದು ಕಂಡು ಬಂದಲ್ಲಿ ನೇಮಕಾತಿಗೆ ಅನರ್ಹರಾಗುತ್ತಾರೆ.
9. ಅರ್ಜಿಯಲ್ಲಿ ತಪ್ಪು ಮಾಹಿತಿ ನೀಡಿ ಉದ್ಯೋಗ ಪಡೆದ ಅಭ್ಯರ್ಥಿಗಳನ್ನು ಯಾವುದೇ ಸಮಯದಲ್ಲಾದರೂ ವಜಾ ಮಾಡಲಾಗುವುದು ಹಾಗೂ ಕಾನೂನಿನ ಕ್ರಮ ಜರುಗಿಸಲಾಗುವುದು.
10. ಅಭ್ಯರ್ಥಿಗಳ ಆಯ್ಕೆಯ ವಿಷಯದಲ್ಲಿ ಆಯ್ಕೆ ಪ್ರಾಧಿಕಾರದ ನಿರ್ಧಾರವೇ ಅಂತಿಮವಾಗಿರುತ್ತದೆ.
11. ಪಿಂಚಣಿ ಸೌಲಭ್ಯ : ಸರ್ಕಾರದ ಆದೇಶ ಸಂಖ್ಯೆ: ಎಫ್‌ಡಿ(ಎಸ್‌ಪಿಎಲ್) 04 ಪಿಇಟಿ 2005, ದಿನಾಂಕ 31.03.2006 ರಂತೆ.
12. ಕೊನೆಯ ದಿನಾಂಕದ ನಂತರ ಸಲ್ಲಿಸಲಾದ ಯಾವುದೇ ಅರ್ಜಿಗಳನ್ನು ಪರಿಗಣಿಸಲಾಗುವುದಿಲ್ಲ. ಅಂಚೆ ಮೂಲಕ ನಿಗದಿತ ದಿನಾಂಕದ ನಂತರ ಬಂದ ಅರ್ಜಿಗಳನ್ನು ಗಣನೆಗೆ ತೆಗೆದುಕೊಳ್ಳಲಾಗುವುದಿಲ್ಲ.
13. ಮೇಲ್ಕಂಡ ಹುದ್ದೆಗಳ ಸಂಖ್ಯೆ ಬದಲಾವಣೆಗೊಳ್ಳುವ ಸಂಭವವಿದೆ.

**ವಿ.ಜಿ. ಸಾವಡ್ಕರ್**
ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಚಾಮರಾಜನಗರ.

**ಅರ್ಜಿ ನಮೂನೆ**

**ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು,**
**ಜಿಲ್ಲಾ ಮತ್ತು ಸತ್ರ ನ್ಯಾಯಾಲಯ, ಚಾಮರಾಜನಗರ.**

**ಇತ್ತೀಚಿನ ಭಾವಚಿತ್ರ ಲಗತ್ತಿಸಿ ಸಹಿ ಮಾಡುವುದು**

**ಮಾನ್ಯರೇ,**

ಚಾಮರಾಜನಗರ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರ ಅಧಿಸೂಚನೆ ಸಂಖ್ಯೆ: ಎಡಿಎಂಎನ್/1875/2013, ದಿನಾಂಕ 02.08.2013 ರ ಪ್ರಕಾರ ಶೀಘ್ರಲಿಪಿಗಾರರ ಹುದ್ದೆಗೆ ನಾನು ಈ ಮೂಲಕ ನನ್ನ ವಿವರದೊಂದಿಗೆ ಅರ್ಜಿ ಸಲ್ಲಿಸಿರುತ್ತೇನೆ.

| | | |
|---|---|---|
| 1 | ಅಭ್ಯರ್ಥಿಯ ಹೆಸರು | |
| 2 | ತಂದೆಯ / ತಾಯಿಯ / ಗಂಡನ ಹೆಸರು | |
| 3 | ಪೂರ್ಣ ವಿಳಾಸ | |
| 4 | ದೂರವಾಣಿ ಸಂಖ್ಯೆ<br>(ಕಡ್ಡಾಯವಾಗಿ ನಮೂದಿಸುವುದು) | |
| 5 | ಜನ್ಮ ದಿನಾಂಕ ಮತ್ತು ವಯಸ್ಸು | |
| 6 | ಲಿಂಗ | ಪುರುಷ / ಮಹಿಳೆ |
| 7 | ವಿವಾಹಿತರಾಗಿದ್ದರೆ ಗಂಡನ ಅಥವ ಹೆಂಡತಿಯ ಹೆಸರು | |
| 8 | ನೀವು ಯಾವ ಮೀಸಲಾತಿಯಡಿ ನೇಮಕಾತಿ ಬಯಸುವಿರಿ<br>( ಕಡ್ಡಾಯವಾಗಿ ನಮೂದಿಸತಕ್ಕದ್ದು) | |
| 9 | ರಾಷ್ಟ್ರೀಯತೆ ಮತ್ತು ಧರ್ಮ | |
| 10 | ಜಾತಿ / ಉಪಜಾತಿ : | |

| | | | | | | |
|---|---|---|---|---|---|---|
| 11 | ಶೈಕ್ಷಣಿಕ ವಿದ್ಯಾರ್ಹತೆಯ ವಿವರಗಳು ಃ (ಸ್ವಯಂ ದೃಢೀಕೃತ ಪ್ರಮಾಣ ಪತ್ರಗಳನ್ನು ಸಲ್ಲಿಸತಕ್ಕದ್ದು) | | | | | |
| | ಉತ್ತೀರ್ಣ ಹೊಂದಿದ ಪರೀಕ್ಷೆಗಳು | ಉತ್ತೀರ್ಣ ಹೊಂದಿದ ವರ್ಷ ಮತ್ತು ನೊಂದಣಿ ಸಂಖ್ಯೆ | ಗರಿಷ್ಠ ಅಂಕಗಳು | ಪಡೆದಿರುವ ಅಂಕಗಳು | ಶೇಕಡಾವಾರು ಅಂಕಗಳು |
| ಎ | ಎಸ್.ಎಸ್.ಎಲ್.ಸಿ. / ತತ್ಸಮಾನ ಪರೀಕ್ಷೆ | | | | |
| ಬಿ | ಹಿರಿಯ ದರ್ಜೆಯ ಕನ್ನಡ ಬೆರಳಚ್ಚು ಪರೀಕ್ಷೆ | | | | |
| ಸಿ | ಹಿರಿಯ ದರ್ಜೆಯ ಆಂಗ್ಲ ಬೆರಳಚ್ಚು ಪರೀಕ್ಷೆ | | | | |
| ಡಿ | ಹಿರಿಯ ದರ್ಜೆಯ ಕನ್ನಡ ಶೀಘ್ರಲಿಪಿ ಪರೀಕ್ಷೆ | | | | |
| ಇ | ಹಿರಿಯ ದರ್ಜೆಯ ಆಂಗ್ಲ ಶೀಘ್ರಲಿಪಿ ಪರೀಕ್ಷೆ | | | | |
| 12 | ಜಾತಿ / ಅಂಗವಿಕಲ/ ಗ್ರಾಮೀಣ ಮೀಸಲಾತಿ ಸೌಲಭ್ಯ ಪಡೆಯ ಬಯಸುವ ಅಭ್ಯರ್ಥಿಗಳು ಸಂಬಂಧಪಟ್ಟ ಅಧಿಕಾರಿಗಳಿಂದ ಪಡೆದ ಪ್ರಮಾಣ ಪತ್ರ ಲಗತ್ತಿಸಬೇಕು | | | | |
| 13 | ನೀವು ಪ್ರಸ್ತುತ ಸರ್ಕಾರಿ ಸೇವೆಯಲ್ಲಿರುವಿರಾ? (ಸರ್ಕಾರಿ ಸೇವೆಯಲ್ಲಿದ್ದಲ್ಲಿ ನೇಮಕಾತಿ ಪ್ರಾಧಿಕಾರದಿಂದ ಪಡೆದ ನಿರಾಕ್ಷೇಪಣ ಪತ್ರದ ನಕಲನ್ನು ಲಗತ್ತಿಸಬೇಕು) | | | | |

**ಸೂಚನೆ ಃ** ಅಭ್ಯರ್ಥಿಯು ತನಗೆ ಅನ್ವಯವಾಗದ್ದನ್ನು ಹೊಡೆದು ಹಾಕತಕ್ಕದ್ದು .

**ಘೋಷಣೆ**

ಈ ಮೇಲೆ ನಮೂದಿಸಿರುವ ಮಾಹಿತಿ ಮತ್ತು ವಿವರಗಳು ನನಗೆ ತಿಳಿದ ಮಟ್ಟಿಗೆ ಸತ್ಯವಾಗಿದ್ದು ಹಾಗೂ ಒಂದು ವೇಳೆ ಅವು ಅಸತ್ಯವೆಂದು ಕಂಡು ಬಂದಲ್ಲಿ ತಾವು ತೆಗೆದುಕೊಳ್ಳುವ ತೀರ್ಮಾನಗಳಿಗೆ ನಾನು ಬದ್ಧನಾಗಿರುತ್ತೇನೆ / ಬದ್ಧಳಾಗಿರುತ್ತೇನೆ. ನಾನು ಆಯ್ಕೆಗೊಂಡರೆ ಚಾಮರಾಜನಗರ ಜಿಲ್ಲಾ ನ್ಯಾಯಾಂಗ ಘಟಕದ ಯಾವುದೇ ನ್ಯಾಯಾಲಯಗಳಲ್ಲಿ ಕರ್ತವ್ಯ ನಿರ್ವಹಿಸಲು ಸಿದ್ದನಿದ್ದೇನೆ / ಸಿದ್ದಳಿದ್ದೇನೆ.

**ಸ್ಥಳ ಃ**

**ದಿನಾಂಕ ಃ** **ಅಭ್ಯರ್ಥಿಯ ಸಹಿ**

**PR.92**

## ಕೋಲಾರ ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರ ಕಛೇರಿ.

### ಅಧಿಸೂಚನೆ ಸಂಖ್ಯೆ ಃ ಎಡಿಎಂ 01/2013 ದಿನಾಂಕಃ 03-08-2013.

**ವಿಷಯ ಃ** ಶೀಘ್ರಲಿಪಿಗಾರರು ಹುದ್ದೆಗಳ ನೇಮಕಾತಿ ಬಗ್ಗೆ.

**ಉಲ್ಲೇಖಃ** 1. ಸರ್ಕಾರಿ ಅಧಿಸೂಚನೆ ಸಂಖ್ಯೆಃ ಎಲ್‌ಎಡಬ್ಲ್ಯೂ 230/ ಎಲ್‌ಸಿಇ-2010, ದಿನಾಂಕಃ 29-03-2011.

2. ಸರ್ಕಾರಿ ಪತ್ರ ಸಂಖ್ಯೆಃ ಎಲ್‌ಎಡಬ್ಲ್ಯೂ 193/ ಎಲ್‌ಎಸಿ-2012, ದಿನಾಂಕಃ 27-08-2012.

3. ಕರ್ನಾಟಕ ಉಚ್ಚ ನ್ಯಾಯಾಲಯ ಬೆಂಗಳೂರು ರವರ ಪತ್ರ ಸಂಖ್ಯೆ ಎಲ್‌ಸಿಎ II 36/2003 ದಿನಾಂಕ 23.06.2011, ಮತ್ತು ಎಲ್‌ಸಿಎ II 128/2012 ದಿನಾಂಕಃ 14.09.2012.

ಕೋಲಾರ ಜಿಲ್ಲೆ, ನ್ಯಾಯಾಂಗ ಇಲಾಖೆಯಲ್ಲಿ ಖಾಲಿ ಇರುವ ಶೀಘ್ರಲಿಪಿಗಾರರ ಹುದ್ದೆಗಳಿಗೆ ಅರ್ಹ ಅಭ್ಯರ್ಥಿಗಳಿಂದ ಈ ಅಧಿಸೂಚನೆಯ ಜೊತೆಗೆ ಲಗತ್ತಿಸಿರುವ ಅರ್ಜಿ ನಮೂನೆಯಲ್ಲಿ ಅರ್ಜಿಗಳನ್ನು ಆಹ್ವಾನಿಸಲಾಗಿದೆ.

**ಅರ್ಜಿಗಳನ್ನು ಸ್ವೀಕರಿಸಲು ಕೊನೆಯ ದಿನಾಂಕ 21-10-2013, ಅಪರಾಹ್ನ 5-00 ಗಂಟೆಯವರೆಗೆ.**

**1. ಶೀಘ್ರಲಿಪಿಗಾರರು ಃ ಖಾಲಿ ಇರುವ ಹುದ್ದೆಗಳು - 09.**

**ವೇತನ ಶ್ರೇಣಿಃ 14550-350-15600-400-17200-450-19000-500-21000-600-24600-700-26700.**

**ಹುದ್ದೆಗಳ ವರ್ಗೀಕರಣ**

| ಮೀಸಲಾತಿ | ಮಹಿಳಾ ಅಭ್ಯರ್ಥಿ | ಗ್ರಾಮೀಣ ಅಭ್ಯರ್ಥಿ | ಕನ್ನಡ ಮಾಧ್ಯಮ | ಇತರೆ | ಒಟ್ಟು ಹುದ್ದೆಗಳು |
|---|---|---|---|---|---|
| ಪ್ರವರ್ಗ-1 | 01 | - | - | - | 01 |
| ಪ್ರವರ್ಗ - 2 (ಎ) | 01 | 01 | - | 01 | 03 |
| ಪ್ರವರ್ಗ - 3 (ಎ) | - | - | - | 01 | 01 |
| ಪ್ರವರ್ಗ - 3 (ಬಿ) | - | - | - | 01 | 01 |
| ಸಾಮಾನ್ಯ | 01 | 01 | 01 | - | 03 |
| ಒಟ್ಟು | 03 | 02 | 01 | 03 | 09 |

**ಶೀಘ್ರಲಿಪಿಗಾರರಿಗೆ ವಿದ್ಯಾರ್ಹತೆ :**

ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆ ಮತ್ತು ಕರ್ನಾಟಕ ಪ್ರೌಢ ಶಿಕ್ಷಣ ಪರೀಕ್ಷಾ ಮಂಡಳಿಯವರು ನಡೆಸುವ ಕನ್ನಡ ಮತ್ತು ಆಂಗ್ಲ ಎರಡೂ ಭಾಷೆಯಲ್ಲೂ ಹಿರಿಯ ಶ್ರೇಣಿ ಬೆರಳಚ್ಚು ಮತ್ತು ಶೀಘ್ರಲಿಪಿ ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಅರ್ಜಿಗಳನ್ನು ಸ್ವೀಕರಿಸಲು ನಿಗಧಿಪಡಿಸಿರುವ ಕಡೆಯ ದಿನಾಂಕದೊಳಗೆ ಉತ್ತೀರ್ಣರಾಗಿರಬೇಕು.

**ಆಯ್ಕೆಯ ವಿಧಾನ :**

ಅರ್ಹತಾ ಪರೀಕ್ಷೆಗಳಲ್ಲಿ ಗಳಿಸಿರುವ ಒಟ್ಟು ಶೇಕಡಾವಾರು ಅಂಕಗಳು ಮತ್ತು ನಿಮಿಷ ಒಂದಕ್ಕೆ 120 ಪದಗಳ ದರದಲ್ಲಿ 5 ನಿಮಿಷಗಳ ಉಕ್ತಲೇಖನವನ್ನು ತೆಗೆದುಕೊಂಡು, ಉಕ್ತಲೇಖನವನ್ನು 45 ನಿಮಿಷಗಳಲ್ಲಿ ಅನುಲಿಪಿ ಮಾಡುವ ಅರ್ಹತಾ ಪರೀಕ್ಷೆಯಲ್ಲಿ ಗಳಿಸುವ ಅಂಕಗಳು ಮತ್ತು ಸಂದರ್ಶನದಲ್ಲಿ ಗಳಿಸುವ ಅಂಕಗಳ ಆಧಾರದ ಮೇಲೆ ಆಯ್ಕೆ ಮಾಡಲಾಗುವುದು.

**ಟಿಪ್ಪಣಿಃ**

ಅರ್ಹತಾ ಪರೀಕ್ಷೆಯು ಗರಿಷ್ಠ 100 ಅಂಕಗಳನ್ನು ಒಳಗೊಂಡಿದ್ದು, ಅದರಲ್ಲಿ ತೇರ್ಗಡೆಯಾಗಲು ಕನಿಷ್ಠ 50 ಅಂಕಗಳನ್ನು ಪಡೆಯಬೇಕು ಮತ್ತು ಸಂದರ್ಶನವು 5 ಅಂಕಗಳನ್ನೊಳಗೊಂಡಿರುತ್ತದೆ.

ಕರ್ನಾಟಕ ಸರ್ಕಾರ ಆದೇಶ ಸಂಖ್ಯೆ ಡಿಪಿಎಆರ್. 59 ಎಸ್.ಸಿ.ಆರ್. 2012 ದಿನಾಂಕ 07.07.2012 ರ ಪ್ರಕಾರ ದಿನಾಂಕ 22.03.2012 ರಿಂದ ಜಾರಿಗೆ ಬಂದಿರುವಂತೆ ಗಣಕಯಂತ್ರ (ಕಂಪ್ಯೂಟರ್) ಜ್ಞಾನ ಕಡ್ಡಾಯ.

ಮಹಿಳಾ ಅಭ್ಯರ್ಥಿಗಳು, ಕನ್ನಡ ಮಾಧ್ಯಮ ಅಭ್ಯರ್ಥಿಗಳು ಹಾಗೂ ಗ್ರಾಮೀಣ ಅಭ್ಯರ್ಥಿಗಳ ಮೀಸಲಾತಿಗಳಲ್ಲಿ ಅರ್ಹ ಅಭ್ಯರ್ಥಿಗಳು ಲಭ್ಯವಿರದೇ ಇದ್ದ ಪಕ್ಷದಲ್ಲಿ, ಆ ಹುದ್ದೆಗಳನ್ನು ಆಯಾ ಪಂಗಡಗಳ ಇತರೆ ಅಭ್ಯರ್ಥಿಗಳಿಂದ ಭರ್ತಿ ಮಾಡಲಾಗುವುದು. ಆಯಾ ಪಂಗಡಗಳ ಇತರೆ ಅಭ್ಯರ್ಥಿಗಳೂ ಸಹ ಲಭ್ಯವಾಗದಿದ್ದಲ್ಲಿ, ಸದರಿ ಹುದ್ದೆಗಳನ್ನು ಸಾಮಾನ್ಯ ಇತರೆ ವರ್ಗದ ಅಭ್ಯರ್ಥಿಗಳಿಂದ ಭರ್ತಿ ಮಾಡಲಾಗುವುದು.

ಅರ್ಹತಾ ಪರೀಕ್ಷೆಗೆ ಹಾಗೂ ಸಂದರ್ಶನಕ್ಕೆ ಆಯ್ಕೆಯಾಗುವ ಅಭ್ಯರ್ಥಿಗಳು ಕೋಲಾರ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರ ಕಛೇರಿಗೆ ತಮ್ಮ ಸ್ವಂತ ಖರ್ಚಿನಲ್ಲಿ ಹಾಜರಾಗತಕ್ಕದ್ದು.

**ವಯೋಮಿತಿಃ**

ಅರ್ಜಿಗಳನ್ನು ಸ್ವೀಕರಿಸಲು ನಿಗದಿಪಡಿಸಿದ ಕೊನೆಯ ದಿನಾಂಕದಂದು ಅಭ್ಯರ್ಥಿಯು

ಅ. ಕನಿಷ್ಠ 18 ವರ್ಷ ವಯಸ್ಸನ್ನು ಪೂರೈಸಿರತಕ್ಕದ್ದು.

ಆ. ಗರಿಷ್ಠ ವಯೋಮಿತಿ

| | |
|---|---|
| ಸಾಮಾನ್ಯ ವರ್ಗ | 35 ವರ್ಷ |
| 2ಎ, 2ಬಿ, 3ಬಿ, 3ಎ | 38 ವರ್ಷ |
| ಪ.ಜಾತಿ, ಪ. ಪಂಗಡ, ಪ್ರವರ್ಗ – 1 | 40 ವರ್ಷ |

ಅಭ್ಯರ್ಥಿಗಳು ಅರ್ಜಿಯನ್ನು ಸಲ್ಲಿಸಲು ನಿಗದಿಪಡಿಸಿದ ಕೊನೆಯ ದಿನಾಂಕದಂದು ಗರಿಷ್ಠ ವಯಸ್ಸನ್ನು ಮೀರಿರಕೂಡದು.

**ವಯೋಮಿತಿ ಸಡಲಿಕೆ :**

ಈ ಕೆಳಗಿನ ಸಂದರ್ಭಗಳಲ್ಲಿ ನೇಮಕಾತಿಯ ಗರಿಷ್ಟ ವಯೋಮಿತಿಯನ್ನು ಆಯಾ ಅಭ್ಯರ್ಥಿಗಳಿಗೆ ನಮೂದಿಸಿರುವ ಮಟ್ಟಿಗೆ ಹೆಚ್ಚಿಸಲಾಗುವುದು.

1. ಅಭ್ಯರ್ಥಿಯು ಕರ್ನಾಟಕ ರಾಜ್ಯ ಸರ್ಕಾರದಲ್ಲಿ ಅಥವಾ ಸ್ಥಳೀಯ ಪ್ರಾಧಿಕಾರದಲ್ಲಿ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಯಾದ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಗೊಂಡು ಕರ್ನಾಟಕ ರಾಜ್ಯ ಸರ್ಕಾರದ ಸ್ವಾಮ್ಯ ಅಥವಾ ನಿಯಂತ್ರಣದಲ್ಲಿರುವ ನಿಗಮದಲ್ಲಿ ಹುದ್ದೆ ಹೊಂದಿರುವ ಅಥವಾ ಹಿಂದೆ ಹೊಂದಿದ್ದಲ್ಲಿ ಗರಿಷ್ಠ ವಯೋಮಿತಿಯನ್ನು ಅವರು ಎಷ್ಟು ವರ್ಷಗಳ ಅವಧಿಗೆ ಹುದ್ದೆಯಲ್ಲಿ ಸೇವೆ ಸಲ್ಲಿಸಿರುವರೋ ಅಥವಾ ಹಿಂದೆ ಸಲ್ಲಿಸಿದ್ದರೋ ಅಷ್ಟು ವರ್ಷಗಳು ಅಥವಾ 10 ವರ್ಷಗಳ ಅವಧಿ, ಎರಡರಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳ ಸಡಿಲಿಕೆಯನ್ನು ನೀಡಲಾಗುವುದು.
2. ಅಭ್ಯರ್ಥಿಯು ಮಾಜಿ ಸೈನಿಕನಾಗಿದ್ದಲ್ಲಿ, ಅವನು ಸಶಸ್ತ್ರ ದಳಗಳಲ್ಲಿ ಎಷ್ಟು ವರ್ಷ ಸೇವೆ ಸಲ್ಲಿಸಿರುವನೋ ಆ ವರ್ಷಗಳಿಗೆ 3 ವರ್ಷಗಳನ್ನು ಸೇರಿಸಿದರೆ ಎಷ್ಟು ವರ್ಷಗಳಾಗುವುದೋ ಅಷ್ಟು ವರ್ಷಗಳು.
3. ಅಭ್ಯರ್ಥಿಯು ವಿಧವೆಯಾಗಿದ್ದಲ್ಲಿ ಮತ್ತು ಜೀತ ಕಾರ್ಮಿಕನಾಗಿದ್ದಲ್ಲಿ 10 ವರ್ಷಗಳು.

**ಪರಿವೀಕ್ಷಣಾ ಅವಧಿ :**

ಆಯ್ಕೆಯಾದ ಅಭ್ಯರ್ಥಿಗಳು ಕರ್ನಾಟಕ ಸೇವಾ ನಿಯಮ (ಪರಿವೀಕ್ಷಣೆ ನಿಯಮಗಳು) 1977ರ ಪ್ರಕಾರ 2 ವರ್ಷಗಳ ಕಾಲ ಪರಿವೀಕ್ಷಣಾ ಅವಧಿಯಲ್ಲಿರುತ್ತಾರೆ. ಈ ಅವಧಿಯಲ್ಲಿ ಅಭ್ಯರ್ಥಿಗಳು ಅವರುಗಳ ಹುದ್ದೆಗೆ ನಿಗದಿಪಡಿಸಿರುವ ಇಲಾಖಾ ಪರೀಕ್ಷೆಗಳಲ್ಲಿ ಮತ್ತು ಕನ್ನಡ ಭಾಷಾ ಪರೀಕ್ಷೆಯಲ್ಲಿ ಉತ್ತೀರ್ಣರಾಗಬೇಕು.

**ಸರ್ಕಾರಿ ಸೇವೆಯಲ್ಲಿರುವ ಅಭ್ಯರ್ಥಿಗಳು ಅರ್ಜಿ ಸಲ್ಲಿಸುವ ವಿಧಾನ :**

ಸರ್ಕಾರಿ ಸೇವೆಯಲ್ಲಿರುವ ಅಭ್ಯರ್ಥಿಗಳು ತಮ್ಮ ನೇಮಕಾತಿ ಪ್ರಾಧಿಕಾರದಿಂದ ನಿರಾಕ್ಷೇಪಣಾ ಪ್ರಮಾಣಪತ್ರವನ್ನು ಪಡೆದು, ಅರ್ಜಿಗಳನ್ನು ಸಂಬಂಧಿತ ನೇಮಕಾತಿ ಪ್ರಾಧಿಕಾರದ ಮೂಲಕ ಕಳುಹಿಸಬೇಕು.

**ಅರ್ಜಿ ಸಲ್ಲಿಸುವ ವಿಧಾನ :**

ಈ ಪ್ರಕಟಣೆಯಲ್ಲಿ ಲಗತ್ತಿಸಿರುವ ಅರ್ಜಿ ನಮೂನೆಯನ್ನು ಬೆರಳಚ್ಚು ಮಾಡಿ/ಕಂಪ್ಯೂಟರ್ ಮೂಲಕ ತಯಾರಿಸಿ, **ಅರ್ಜಿಯನ್ನು ತಮ್ಮ ಸ್ವಂತ ಕೈಬರಹದಲ್ಲಿ ತಮಗೆ ಅನ್ವಯಿಸುವ ಎಲ್ಲಾ ಅಂಕಣಗಳನ್ನು ಭರ್ತಿ ಮಾಡುವುದು.**_ ಅಭ್ಯರ್ಥಿಯು ತನ್ನ ಇತ್ತೀಚಿನ ಪಾಸ್‌ಪೋರ್ಟ್ ಅಳತೆಯ ಭಾವಚಿತ್ರವನ್ನು ಅರ್ಜಿಯ ಮೇಲೆ ಅಂಟಿಸಿ, ಅದರ ಮೇಲೂ ಸಹ ಸಹಿ ಮಾಡುವುದು ಹಾಗೂ ಅರ್ಜಿ ನಮೂನೆಯ ಕೊನೆಯಲ್ಲಿ ಘೋಷಣೆಯ ನಂತರ ಸಹಿ ಮಾಡುವುದು. ಹುದ್ದೆಗೆ ಸಂಬಂಧಿಸಿದಂತೆ ವಿದ್ಯಾರ್ಹತೆ, ವಯಸ್ಸು ಮತ್ತು ಕೋರಿರುವ ಮೀಸಲಾತಿಗೆ ಸಂಬಂಧಿಸಿದಂತೆ ಪ್ರಮಾಣ ಪತ್ರಗಳನ್ನು ಅಧಿಕೃತ

ಅಧಿಕಾರಿಗಳಿಂದ ಪಡೆದು, ಅವುಗಳ ನಕಲುಗಳನ್ನು ಸ್ವಯಂ ಧೃಢೀಕರಿಸಿ ಅರ್ಜಿಯೊಂದಿಗೆ ಲಗತ್ತಿಸಿ ಅರ್ಜಿಯನ್ನು **'ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಜಿಲ್ಲಾ ಮತ್ತು ಸತ್ರ ನ್ಯಾಯಾಲಯ, ಕೋಲಾರ – 563101'**, ಇವರಿಗೆ ದಿನಾಂಕ : 21–10–2013 ಅಪರಾಹ್ನ 5–00 ಗಂಟೆಯೊಳಗೆ ತಲುಪುವಂತೆ ಕಳುಹಿಸುವುದು.

**ಅಭ್ಯರ್ಥಿಗಳು ಅರ್ಜಿಯೊಂದಿಗೆ ಲಗತ್ತಿಸಬೇಕಾದ ದಾಖಲಾತಿಗಳು:**

ಅಭ್ಯರ್ಥಿಗಳು ಈ ಕೆಳಕಂಡ ದಾಖಲಾತಿಗಳ ಸ್ವಯಂ ಧೃಢಿಕರಿಸಿದ ಒಂದು ಪ್ರತಿಯನ್ನು ಅರ್ಜಿಯೊಂದಿಗೆ ಲಗತ್ತಿಸಬೇಕು.

1. ಇತ್ತಿಚಿನ ಪಾಸ್‌ಪೋರ್ಟ್ ಅಳತೆಯ ಭಾವಚಿತ್ರ.
2. ಜನ್ಮ ದಿನಾಂಕದ ಧೃಡೀಕರಣಕ್ಕಾಗಿ ಎಸ್‌ಎಸ್‌ಎಲ್‌ಸಿ ಅಂಕ ಪಟ್ಟಿ/ಕ್ಯುಮುಲೇಟೀವ್ ರೆಕಾರ್ಡ್/ಇನ್ನಾವುದೇ ಅಧಿಕೃತ ದಾಖಲಾತಿಗಳು.
3. ವಿದ್ಯಾರ್ಹತೆಯ ಬಗ್ಗೆ ಅಂಕಪಟ್ಟಿಗಳು.
4. ಪ್ರವರ್ಗ–1 ರ ಅಭ್ಯರ್ಥಿಗಳು ನಮೂನೆ –ಇ ಯಲ್ಲಿ ಮತ್ತು 2–ಎ , 3–ಎ ಮತ್ತು 3–ಬಿ ಗೆ ಸೇರಿದ ಅಭ್ಯರ್ಥಿಗಳು ನಮೂನೆ 'ಎಫ್'ನಲ್ಲಿ ಸಂಬಂಧಿಸಿದ ತಹಶೀಲ್ದಾರರಿಂದ ಜಾತಿ ಮತ್ತು ಆದಾಯ ಪ್ರಮಾಣ ಪತ್ರಗಳನ್ನು ಪಡೆದು ಸಲ್ಲಿಸಬೇಕು.
5. ಗ್ರಾಮೀಣ ಮೀಸಲಾತಿಯನ್ನು ಕೋರುವ ಅಭ್ಯರ್ಥಿಗಳು ನಿಗದಿತ ನಮೂನೆ – 2 ರಲ್ಲಿ ಅಧಿಕೃತ ಅಧಿಕಾರಿಗಳಿಂದ ಪಡೆದು ಅದನ್ನು ಸಂಬಂಧಿಸಿದ ಕ್ಷೇತ್ರ ಶಿಕ್ಷಣಾಧಿಕಾರಿಗಳಿಂದ ಮೇಲು ಸಹಿ ಮಾಡಿಸಿ ಸಲ್ಲಿಸಬೇಕು.
6. ಗ್ರಾಮೀಣ ಮೀಸಲಾತಿಯನ್ನು ಕೋರುವ ಸಾಮಾನ್ಯ ವರ್ಗದ ಅಭ್ಯರ್ಥಿಗಳು ಪ್ರಮಾಣ ಪತ್ರ ನಮೂನೆ – 2 ರ ಜೊತೆ ನಮೂನೆ – 1 ರಲ್ಲೂ ಧೃಢಿಕರಣ ಪತ್ರವನ್ನು ಸಲ್ಲಿಸುವುದು.
7. ವಿಧವೆಯರು, ಜೀತ ಕಾರ್ಮಿಕರು ವಯೋಮಿತಿ ರಿಯಾಯ್ತಿ ಕೋರಲು ಸಕ್ಷಮ ಪ್ರಾಧಿಕಾರದಿಂದ ಪಡೆದ ಪ್ರಮಾಣಪತ್ರವನ್ನು ಸಲ್ಲಿಸುವುದು.
8. ಅರ್ಜಿಯನ್ನು ಕಳುಹಿಸಲು ನಿಗದಿಪಡಿಸಿದ ದಿನಾಂಕದಂದು 6 ತಿಂಗಳ ಒಳಗೆ ಇಬ್ಬರು ಗೌರವಾನ್ವಿತ ವ್ಯಕ್ತಿಗಳು ನೀಡಿರುವ ನಡತೆ ಪ್ರಮಾಣಪತ್ರವನ್ನು ಸಲ್ಲಿಸುವುದು.
9. ಸ್ವಯಂ ವಿಳಾಸವಿರುವ ರೂ 5/– ಅಂಚೆ ಚೀಟಿ ಅಂಟಿಸಿರುವ ಲಕೋಟೆಯನ್ನು ಅರ್ಜಿಯೊಂದಿಗೆ ಲಗತ್ತಿಸುವುದು.

**ವಿಶೇಷ ಸೂಚನೆ:**

ಅಭ್ಯರ್ಥಿಗಳು ಒಂದಕ್ಕಿಂತ ಹೆಚ್ಚಿನ ಮೀಸಲಾತಿಯನ್ನು ಕೋರಿದ್ದಲ್ಲಿ, ಪ್ರತ್ಯೇಕ ಮೀಸಲಾತಿಗಾಗಿ ಪ್ರತ್ಯೇಕ ಅರ್ಜಿಯನ್ನು ಸಲ್ಲಿಸತಕ್ಕದ್ದು. ಒಂದೇ ಅರ್ಜಿಯಲ್ಲಿ ಒಂದಕ್ಕಿಂತ ಹೆಚ್ಚಿನ ಮೀಸಲಾತಿಯನ್ನು ಕೋರಿದಲ್ಲಿ, ಅಂತಹ ಅರ್ಜಿಗಳನ್ನು ಯಾವುದೇ ಕಾರಣವಿಲ್ಲದೇ ತಿರಸ್ಕರಿಸಲಾಗುವುದು.

ಅರ್ಜಿಯೊಂದಿಗೆ ಲಗತ್ತಿಸುವ ಎಲ್ಲಾ ಪ್ರಮಾಣಪತ್ರಗಳು ಅರ್ಜಿ ಸಲ್ಲಿಸಲು ನಿಗದಿಪಡಿಸಿರುವ ಕೊನೆಯ ದಿನಾಂಕದೊಳಗೆ ಪಡೆದಿರಬೇಕು ಇಲ್ಲವೇ ಕೊನೆಯ ದಿನಾಂಕದಂದು ಸಿಂಧುವಾಗಿರಬೇಕು ಮತ್ತು ಕಡ್ಡಾಯವಾಗಿ ಸ್ವಯಂ ಧೃಢೀಕರಿಸಿರಬೇಕು.

ಯಾವುದೇ ಅಭ್ಯರ್ಥಿಯು ಸರ್ಕಾರಿ/ಸರ್ಕಾರೇತರ ಅಧಿಕಾರಿಗಳಿಂದ ತನ್ನ ಅಭ್ಯರ್ಥಿತ್ವದ ಬಗ್ಗೆ ಪ್ರಭಾವ ಬೀರಿದರೆ ಅಂತಹ ಅಭ್ಯರ್ಥಿಗಳು ನೇಮಕಾತಿಗೆ ಅರ್ಹರಾಗಿರುವುದಿಲ್ಲ.

ಯಾವುದೇ ಅಭ್ಯರ್ಥಿಯು ಸಂದರ್ಶನದ ಬಗ್ಗೆ ಮಾಹಿತಿ ಬರದಿದ್ದರೆ, ಅವರು ಸಂದರ್ಶನಕ್ಕೆ ಅರ್ಹರಲ್ಲ ಎಂದು ತಿಳಿಯುವುದು ಮತ್ತು ಈ ಬಗ್ಗೆ ಯಾವುದೇ ಪತ್ರ ವ್ಯವಹಾರವನ್ನು ಮಾಡಲಾಗುವುದಿಲ್ಲ.

ಅರ್ಜಿಗಳನ್ನು ಸ್ವೀಕರಿಸಲು ನಿಗದಿಪಡಿಸಿದ ಕೊನೆಯ ದಿನಾಂಕವು ಸಾರ್ವಜನಿಕ ರಜೆಯಾಗಿದ್ದರೆ ಮುಂದಿನ ಕಛೇರಿ ಕೆಲಸದ ದಿನ ಅರ್ಜಿ ಸಲ್ಲಿಸಲು ಕಡೆಯ ದಿನಾಂಕ ಎಂದು ತಿಳಿಯುವುದು.

**ಎಸ್.ರೇಣುಕಾ ಪ್ರಸಾದ್**

ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಕೋಲಾರ.

**ಅರ್ಜಿ ನಮೂನೆ**

| ಅಭ್ಯರ್ಥಿಯ ಇತ್ತೀಚಿನ ಪಾಸ್‌ಪೋರ್ಟ್ ಅಳತೆಯ ಭಾವಚಿತ್ರದ ಮೇಲೆ ಸಹಿ ಮಾಡಿ ಅಂಟಿಸುವುದು |
|---|

ರವರಿಗೆ,

ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು,

ಕೋಲಾರ.

ತಮ್ಮ ಕಛೇರಿಯ ಅಧಿಸೂಚನೆ ಸಂಖ್ಯೆ ಎಡಿಎಂ/01/2013, ದಿನಾಂಕ: 03–08–2013 ರ ಮೇರೆಗೆ ನಾನು ಶೀಘ್ರಲಿಪಿಗಾರರ ಹುದ್ದೆಗೆ ಅರ್ಜಿಯನ್ನು ಸಲ್ಲಿಸುತ್ತಿದ್ದೇನೆ ಮತ್ತು ಈ ಕೆಳಕಂಡ ಮಾಹಿತಿಯನ್ನು ಒದಗಿಸುತ್ತಿದ್ದೇನೆ.

| | | | | |
|---|---|---|---|---|
| 1 | ಅಭ್ಯರ್ಥಿಯ ಹೆಸರು (ದಪ್ಪ ಅಕ್ಷರಗಳಲ್ಲಿ) | | | |
| 2 | ತಂದೆ/ಗಂಡನ ಹೆಸರು | | | |
| 3 | ತಾಯಿಯ ಹೆಸರು | | | |
| 4 | ಜನ್ಮ ದಿನಾಂಕ | | | |
| 5 | ವಯಸ್ಸು (ಅರ್ಜಿಯನ್ನು ಸ್ವೀಕರಿಸಲು ನಿಗದಿಪಡಿಸಿರುವ ಕೊನೆ ದಿನಾಂಕದಂದು ಅಭ್ಯರ್ಥಿ ವಯಸ್ಸು) | ವರ್ಷ | ತಿಂಗಳು | ದಿನ |
| | | | | |
| 6 | ಲಿಂಗ | ಪುರುಷ | | ಮಹಿಳೆ |
| | | | | |
| 7 | ರಾಷ್ಟ್ರೀಯತೆ | | | |
| 8 | ಧರ್ಮ ಮತ್ತು ಜಾತಿ | | | |

| | | | | |
|---|---|---|---|---|
| 9 | ವೈವಾಹಿಕ ಸ್ಥಿತಿ | ವಿವಾಹಿತ | | ಅವಿವಾಹಿತ |
| | | | | |
| 10 | ಕೋರುವ ಮೀಸಲಾತಿಗಳು (ಸಾಮಾನ್ಯ, 2ಎ, 3ಎ, 3ಬಿ, ಪ್ರವರ್ಗ-1) ಮೀಸಲಾತಿಯನ್ನು ಸ್ಪಷ್ಟವಾಗಿ ನಮೂದಿಸತಕ್ಕದ್ದು ಮತ್ತು ಪ್ರಮಾಣ ಪತ್ರದ ಸ್ವಯಂ ಧೃಡೀಕೃತ ನಕಲನ್ನು ಲಗತ್ತಿಸಬೇಕು) | | | |
| 11 | ನೀವು ಈ ಯಾವುದಾದರು ಮೀಸಲಾತಿ ಅಡಿಯಲ್ಲಿ ಬರುತ್ತೀರಾ? (ಗ್ರಾಮೀಣ, ಕನ್ನಡ ಮಾಧ್ಯಮ ಅಭ್ಯರ್ಥಿ) ಮೀಸಲಾತಿಯನ್ನು ಸ್ಪಷ್ಟವಾಗಿ ನಮೂದಿಸತಕ್ಕದ್ದು ಮತ್ತು ಪ್ರಮಾಣ ಪತ್ರದ ಸ್ವಯಂ ಧೃಡೀಕೃತ ನಕಲನ್ನು ಲಗತ್ತಿಸಬೇಕು) | | | |
| 12 | **ವಿದ್ಯಾರ್ಹತೆ :**<br>(ಸ್ವಯಂ ಧೃಢಿಕೃತ ಪ್ರಮಾಣ ಪತ್ರಗಳನ್ನು ಸಲ್ಲಿಸತಕ್ಕದ್ದು) | ತೇರ್ಗಡೆಯಾದ ತಿಂಗಳು ಮತ್ತು ವರ್ಷ | ಗರಿಷ್ಠ ಅಂಕಗಳು | ಗಳಿಸಿದ ಅಂಕಗಳು |
| | ಎಸ್.ಎಸ್.ಎಲ್.ಸಿ; | | | |
| | ಕನ್ನಡ ಬೆರಳಚ್ಚು (ಹಿರಿಯ ಶ್ರೇಣಿ) | | | |
| | ಆಂಗ್ಲ ಬೆರಳಚ್ಚು (ಹಿರಿಯ ಶ್ರೇಣಿ) | | | |
| | ಕನ್ನಡ ಶೀಘ್ರಲಿಪಿ (ಹಿರಿಯ ಶ್ರೇಣಿ) | | | |
| | ಆಂಗ್ಲ ಶೀಘ್ರಲಿಪಿ (ಹಿರಿಯ ಶ್ರೇಣಿ) | | | |
| | ಇತರೆ ಯಾವುದೇ ವಿದ್ಯಾರ್ಹತೆ | | | |
| 13 | ನೀವು ಪ್ರಸ್ತುತ ಸರ್ಕಾರಿ ಸೇವೆಯಲ್ಲಿರುವಿರಾ? (ಸರ್ಕಾರಿ ಸೇವೆಯಲ್ಲಿದ್ದಲ್ಲಿ ನೇಮಕಾತಿ ಪ್ರಾಧಿಕಾರದಿಂದ ಪಡೆದ ನಿರಾಕ್ಷೇಪಣಾ ಪತ್ರದ ನಕಲನ್ನು ಲಗತ್ತಿಸಬೇಕು) | ಹೌದು | | ಇಲ್ಲ |
| 14 | ಅಭ್ಯರ್ಥಿಯ ಅಂಚೆ ವಿಳಾಸ ಮತ್ತು ದೂರವಾಣಿ ಸಂಖ್ಯೆ | | | |
| 15 | ನಿಮ್ಮ ಸ್ವವಿಳಾಸವಿರುವ ರೂ.5/- ರ ಅಂಚೆ ಚೀಟಿ ಅಂಟಿಸಿರುವ ಲಕೋಟೆಯನ್ನು ಲಗತ್ತಿಸಿದ್ದೀರ? | | | |

ಈ ಮೇಲ್ಕಂಡ ಮಾಹಿತಿಗಳು ಸತ್ಯವಾಗಿರುತ್ತದೆ ಎಂದು ಪ್ರಮಾಣೀಕರಿಸುತ್ತೇನೆ ಹಾಗೂ ಒಂದು ವೇಳೆ ಮೇಲ್ಕಂಡ ಮಾಹಿತಿಗಳು ತಪ್ಪು ಎಂದು ಕಂಡು ಬಂದಲ್ಲಿ ನನ್ನ ಅಭ್ಯರ್ಥಿತ್ವವನ್ನು ರದ್ದುಪಡಿಸಬಹುದೆಂದು ಘೋಷಿಸುತ್ತೇನೆ.

ಸ್ಥಳ :

ದಿನಾಂಕ: ಅಭ್ಯರ್ಥಿಯ ಸಹಿ.

**PR.93**
**SC.5**

**ಆಯುಷ್ ಇಲಾಖೆ ಆಯುಷ್ ನಿರ್ದೇಶನಾಲಯ, ಧನ್ವಂತರಿ ರಸ್ತೆ, ಬೆಂಗಳೂರು-560 009**

**ಸಂಖ್ಯೆ: ಆಯುಷ್/170/ಸಿ(2)/2012-13, ದಿ: 31-08-2013**

**ಅಧಿಸೂಚನೆ**

**"ಶುಶ್ರೂಷಕಿ ಮತ್ತು ಔಷಧ ವಿತರಕರು ಹುದ್ದೆಗಳಿಗೆ ಬ್ಯಾಕ್ ಲಾಗ್ ನೇರ ನೇಮಕಾತಿ"**

**"ಪರಿಶಿಷ್ಟ ಜಾತಿ/ಪರಿಶಿಷ್ಠ ಪಂಗಡದ ಅಭ್ಯರ್ಥಿಗಳು ಮಾತ್ರ ಅರ್ಜಿ ಸಲ್ಲಿಸಬೇಕು"**

ಸರ್ಕಾರಿ ಅಧಿಸೂಚನೆ ಸಂಖ್ಯೆ: ಡಿಪಿಎಆರ್/13/ಎಸ್‌ಬಿಸಿ.2001 ದಿ: 21-11-2001 ಕ್ಕೆ ಅನುಗುಣವಾಗಿ ಆಯುಷ್ ಇಲಾಖೆಯಲ್ಲಿ ಅರೆ ವೈದ್ಯಕೀಯ ಗ್ರೂಪ್-ಸಿ ವೃಂದದ ಶುಶ್ರೂಷಕಿ ಮತ್ತು ಔಷಧ ವಿತರಕರು ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡಗಳಿಗೆ ಮೀಸಲಿರಿಸಿದ್ದ ಹಾಗೂ ಭರ್ತಿಯಾಗದೆ ಖಾಲಿ ಉಳಿದಿರುವ ಹುದ್ದೆಗಳು (ವಿಶೇಷ ನೇಮಕಾತಿ) ನಿಯಮಗಳು 2001 ರಲ್ಲಿ ನಿಗದಿಪಡಿಸಿರುವಂತೆ ಅರ್ಹತೆ ಮತ್ತು ಮೀಸಲಾತಿ ಆಧಾರದ ಮೇಲೆ ಈ ಕೆಳಕಂಡ ಬ್ಯಾಕ್ ಲಾಗ್ ಹುದ್ದೆಗಳಿಗೆ ಅರ್ಜಿಯನ್ನು ಆಹ್ವಾನಿಸಲಾಗಿದೆ.

**"ಶುಶ್ರೂಷಕಿ -05 ಹುದ್ದೆಗಳು**

| **ಕ್ರ.ಸಂ.** | **ಮೀಸಲಾತಿ** | | | | | | **ವಯೋಮಿತಿ** |
|---|---|---|---|---|---|---|---|
| | | ಸಾಮಾನ್ಯ ಅಭ್ಯರ್ಥಿ (ಇತರೆ) | ಮಹಿಳೆ | ಗ್ರಾಮೀಣ | ಅಂಗವಿಕಲ | ಒಟ್ಟು | ಕನಿಷ್ಠ - 18, ಗರಿಷ್ಠ - 40 |
| 1 | ಪರಿಶಿಷ್ಟ ಪಂಗಡ | 01 | 02 | 01 | 01 | 05 | |

**ಔಷಧ ವಿತರಕರು –09 ಹುದ್ದೆಗಳು**

| ಕ್ರ.ಸಂ. | ಮೀಸಲಾತಿ | | | | | | ವಯೋಮಿತಿ |
|---|---|---|---|---|---|---|---|
| | | ಸಾಮಾನ್ಯ ಅರ್ಹತೆ (ಇತರೆ) | ಮಹಿಳೆ | ಗ್ರಾಮೀಣ | ಅಂಗವಿಕಲ | ಒಟ್ಟು | ಕನಿಷ್ಠ – 18, ಗರಿಷ್ಠ – 40 |
| 1 | ಪರಿಶಿಷ್ಟ ಜಾತಿ | 02 | 03 | 03 | 01 | 09 | |

**ಸೂಚನೆ:**

→ ಅರ್ಜಿಯನ್ನು ವೆಬ್‌ಸೈಟ್ ವಿಳಾಸ **www.karunadu/ayush.gov.in** ಮುಖಾಂತರ ಆಹ್ವಾನಿಸಲಾಗಿದೆ. ವೆಬ್‌ಸೈಟ್‌ನಲ್ಲಿ ಅರ್ಜಿಗಳನ್ನು ಭರ್ತಿ ಮಾಡುವುದು, ನಂತರ ಒಂದು ಅರ್ಜಿಯುನ್ನು ಡೌನ್‌ಲೋಡ್ ಮುಖಾಂತರ ಪಡೆದು ಅಭ್ಯರ್ಥಿಯ ಫೋಟೋ ಮತ್ತು ಸಹಿ ಮಾಡಿ ಸದರಿ ಅರ್ಜಿಯನ್ನು ಅಭ್ಯರ್ಥಿಯು ಸ್ವಂತ ಬರವಣಿಗೆಯಲ್ಲಿ ಭರ್ತಿ ಮಾಡುವುದು.

→ ಭರ್ತಿ ಮಾಡಿದ ಅರ್ಜಿಯನ್ನು ನೇರವಾಗಿ ನಿರ್ದೇಶಕರು, ಆಯುಷ್ ನಿರ್ದೇಶನಾಲಯ, ಧನ್ವಂತರಿ ರಸ್ತೆ, ಬೆಂಗಳೂರು–560 009, ಇಲ್ಲಿಗೆ **ರೂ.ಇಪ್ಪತ್ತೈದು** ಡಿಡಿಯನ್ನು ಆಡಳಿತಾಧಿಕಾರಿಗಳು, ಆಯುಷ್ ನಿರ್ದೇಶನಾಲಯ, ಬೆಂಗಳೂರು, ರವರ ಹೆಸರಿಗೆ ಪಡೆದು ಲಗತ್ತಿಸಿ ನೊಂದಾಯಿತ ಅಂಚೆ ಮೂಲಕ ಸಲ್ಲಿಸುವುದು.

✷ ಅರ್ಜಿ ಸಲ್ಲಿಸಲು ಪ್ರಾರಂಭ ದಿನಾಂಕ: 10–09–2013

✷ ಶುಲ್ಕದೊಂದಿಗೆ ಅರ್ಜಿ ಸಲ್ಲಿಸಲು ಕೊನೆಯ ದಿನಾಂಕ: 23–10–2013

**ಟಿಪ್ಪಣಿ:** ಅನುಸೂಚಿಯಲ್ಲಿ ತಿಳಿಸಿರುವ ಹುದ್ದೆಗಳ ವರ್ಗೀಕರಣವು ಅನಿವಾರ್ಯ ಸಂದರ್ಭದಲ್ಲಿ ಬದಲಾವಣೆಗೆ ಒಳಪಟ್ಟಿರುತ್ತದೆ

1. **ಅರ್ಹತಾ ಷರತ್ತುಗಳು:**

ಅ) ಭಾರತೀಯ ನಾಗರೀಕನಾಗಿರತಕ್ಕದ್ದು

ಆ) ಒಬ್ಬ ಜೀವಂತ ಪತ್ನಿಗಿಂತ ಹೆಚ್ಚು ಮಂದಿ ಪತ್ನಿಯರನ್ನು ಹೊಂದಿರುವ ಪುರುಷ ಅಭ್ಯರ್ಥಿ ಮತ್ತು ಈಗಾಗಲೇ ಇನ್ನೊಬ್ಬ ಹೆಂಡತಿರುವ ವ್ಯಕ್ತಿಯನ್ನು ಮದುವೆಯಾಗಿರುವ ಮಹಿಳಾ ಅಭ್ಯರ್ಥಿಯು ಸರ್ಕಾರದಿಂದ ಪೂರ್ವಾನುಮತಿಯನ್ನು ಪಡೆಯದೇ ನೇಮಕಾತಿಗೆ ಅರ್ಹರಾಗುವುದಿಲ್ಲ.

ಇ) ಅಭ್ಯರ್ಥಿಯು ಮಾನಸಿಕವಾಗಿ ಮತ್ತು ದೈಹಿಕವಾಗಿ ಆರೋಗ್ಯವಂತರಾಗಿರಬೇಕು ಮತ್ತು ಅವರ ನೇಮಕಾತಿಯು ಕರ್ತವ್ಯಗಳ ದಕ್ಷ ನಿರ್ವಹಣೆಗೆ ಆತಂಕವನ್ನುಂಟು ಮಾಡುವ ಸಂಭವ ಇರುವ ಯಾವುದೇ ದೈಹಿಕ ನ್ಯೂನತೆಯಿಂದ ಮುಕ್ತರಾಗಿರಬೇಕು.

ಈ) ದೈಹಿಕವಾಗಿ ಅನರ್ಹರಾಗಿದ್ದಾರೆಂಬುದಾಗಿ ವೈದ್ಯಕೀಯ ಮಂಡಳಿಯ ವರದಿಯ ಮೇಲೆ ಅನರ್ಹರೆಂಬುದಾಗಿ ತಿರಸ್ಕರಿಸುವ ಪೂರ್ಣ ವಿವೇಚನೆಯನ್ನು ರಾಜ್ಯ ಸರ್ಕಾರವು ಕಾದಿರಿಸಿಕೊಂಡಿದೆ ಮತ್ತು ಸರ್ಕಾರದ ವಿವೇಚನೆಯು ಯಾವುದೇ ವಿಧದಲ್ಲೂ ಈ ನಿಯಮಗಳ ಮೂಲಕ ಸೀಮಿತವಾಗಿರುವುದಿಲ್ಲ.

ಉ) ನಿಗದಿತ ಶೈಕ್ಷಣಿಕ ಅರ್ಹತೆಯ ಜೊತೆಗೆ ಈ ಮೇಲ್ಕಂಡ ಅರ್ಹತೆಗಳನ್ನು ಹೊಂದಿರುವ ಅಭ್ಯರ್ಥಿಗಳು ನೇಮಕಾತಿಗಾಗಿ ಅರ್ಜಿ ಸಲ್ಲಿಸಲು ಅರ್ಹತೆಯನ್ನು ಹೊಂದಿರುತ್ತಾರೆ.

* ಪದನಾಮ, ವೇತನ ಶ್ರೇಣಿ, ಹುದ್ದೆಗಳ ಸಂಖ್ಯೆ, ನಿಗದಿಪಡಿಸಿರುವ ವಿದ್ಯಾರ್ಹತೆ, ತರಬೇತಿ ಮತ್ತು ವಯೋಮಿತಿ ವಿವರ ಈ ಕೆಳಕಂಡಂತೆ

| ಕ್ರ.ಸಂ | ಹುದ್ದೆಯ ಪದನಾಮ ವೇತನ ಶ್ರೇಣಿ ಮತ್ತು ಒಟ್ಟು ಹುದ್ದೆಗಳು | ವೇತನ ಶ್ರೇಣಿ | ನಿಗದಿಪಡಿಸಿರುವ ಕನಿಷ್ಠ ವಿದ್ಯಾರ್ಹತೆ | ವಯೋಮಿತಿ ಮತ್ತು ಆಯ್ಕೆವಿಧಾನ |
|---|---|---|---|---|
| 1 | ಶುಶ್ರೂಷಕರು (ಪರಿಶಿಷ್ಟ ಪಂಗಡ ಹುದ್ದೆ–05) | ರೂ.17650–32000 | Must have passed in SSLC or equivalent Qualification with Diploma in Nursing 3 ½ years course of an institution recognized by the Govt. of Karnataka. | ಎಸ್.ಎಸ್.ಎಲ್.ಸಿ. ಯಲ್ಲಿ ಒಟ್ಟು ಶೇಕಡವಾರು + ನರ್ಸಿಂಗ್ ಡಿಪ್ಲೊಮದಲ್ಲಿ ಪಡೆದ ಒಟ್ಟು ಶೇಕಡವಾರು =ಒಟ್ಟು 2ರಲ್ಲಿ ಭಾಗಿಸಿ =% |
| 2 | ಔಷಧ ವಿತರಕರು (ಪರಿಶಿಷ್ಟ ಜಾತಿ ಹುದ್ದೆ–09) | ರೂ.14550–26700 | Must be holder of Diploma in Pharmacy (AYUSH) from a recognized institution.<br>Provided that if no candidates is available then a candidate who passed PUC with Science subject or equivalent qualification and Diploma in Pharmacy from institution recognized by Government of Karnataka. | ಪಿ.ಯು.ಸಿ. ಯಲ್ಲಿ ಒಟ್ಟು ಶೇಕಡವಾರು + ಫಾರ್ಮಸಿ ಡಿಪ್ಲೊಮದಲ್ಲಿ ಪಡೆದ ಒಟ್ಟು ಶೇಕಡವಾರು =ಒಟ್ಟು 2ರಲ್ಲಿ ಭಾಗಿಸಿ =% |

**2.ವಯೋಮಿತಿ:** ಭರ್ತಿ ಮಾಡಿದ ಅರ್ಜಿಗಳನ್ನು ಸ್ವೀಕರಿಸಲು ಕೊನೆಯ ದಿನಾಂಕಕ್ಕೆ ಕನಿಷ್ಠ 18 ವರ್ಷಗಳು ಗರಿಷ್ಠ 40 ವರ್ಷಗಳನ್ನು ಮೀರಿರಬಾರದು. ವಿಶೇಷ ನೇಮಕಾತಿ ನಿಯಮಗಳನ್ವಯ 29 ವರ್ಷ ಪೂರ್ಣಗೊಳಿಸಿರುವ ಅಭ್ಯರ್ಥಿಗಳನ್ನು ಮಾತ್ರ ಆಯ್ಕೆಗೆ ಪರಿಗಣಿಸಲಾಗುವುದು. 29 ರಿಂದ 40 ವರ್ಷಗಳ ವಯಸ್ಸಿನ ಅಭ್ಯರ್ಥಿಗಳು ಲಭ್ಯವಿಲ್ಲದಿದ್ದಾಗ ಮಾತ್ರ 18 ರಿಂದ 29 ವರ್ಷ ವಯಸ್ಸಿನ ಅಭ್ಯರ್ಥಿಗಳನ್ನು ಪರಿಗಣಿಸಲಾಗುವುದು.

**3.ಶೈಕ್ಷಣಿಕ ವಿದ್ಯಾರ್ಹತೆ:** ಅರ್ಜಿಗಳನ್ನು ಭರ್ತಿ ಮಾಡಲು ನಿಗದಿಪಡಿಸಿದ ಕೊನೆಯ ದಿನಾಂಕದಂದು ಅನುಸೂಚಿಯಲ್ಲಿ ಅಧಿಸೂಚಿಸಿದ ಹುದ್ದೆಯ ಮುಂದೆ ಸೂಚಿಸಿರುವ ವಿದ್ಯಾರ್ಹತೆಯನ್ನು ಅಭ್ಯರ್ಥಿಗಳು ಕಡ್ಡಾಯವಾಗಿ ಹೊಂದಿರಬೇಕು. ಹುದ್ದೆಗೆ ನಿಗದಿಪಡಿಸಿರುವ ವಿದ್ಯಾರ್ಹತೆಯನ್ನು ಅಭ್ಯರ್ಥಿಗಳು ಅರ್ಜಿಯಲ್ಲಿ ಸ್ಪಷ್ಟವಾಗಿ ನಮೂದಿಸಬೇಕು.

**4.ಜಾತಿ / ಮೀಸಲಾತಿ ಪ್ರಮಾಣ ಪತ್ರಗಳು:** ಮೀಸಲಾತಿ ಕೋರಬಯಸುವ ಅಭ್ಯರ್ಥಿಗಳು ಈ ಕೆಳಗೆ ನಮೂದಿಸಿರುವ ನಮೂನೆಗಳಲ್ಲಿಯೇ ಮೀಸಲಾತಿ ಪ್ರಮಾಣ ಪತ್ರಗಳನ್ನು ಸಲ್ಲಿಸತಕ್ಕದ್ದು: ಅರ್ಜಿ ಸಲ್ಲಿಸಲು ನಿಗದಿಪಡಿಸಿದ ಕೊನೆ ದಿನಾಂಕದೊಳಗೆ ಚಾಲ್ತಿಯಲ್ಲಿರುವ ಮೀಸಲಾತಿ ಪ್ರಮಾಣ ಪತ್ರವನ್ನು ಸಂಬಂಧಿತ ತಹಸೀಲ್ದಾರ್‌ರವರಿಂದ ಪಡೆದಿಟ್ಟುಕೊಂಡಿರತಕ್ಕದ್ದು. ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ತಪ್ಪದೇ ಹಾಜರುಪಡಿಸತಕ್ಕದ್ದು, ತಪ್ಪಿದಲ್ಲಿ ಅಂತಹ ಅಭ್ಯರ್ಥಿಗಳ ಮೀಸಲಾತಿಯನ್ನು ರದ್ದುಪಡಿಸಲಾಗುವುದು. ಈ ಪ್ರಮಾಣ ಪತ್ರಗಳ ನಮೂನೆಗಳನ್ನು ಈ ಸೂಚನೆಗಳಲ್ಲಿ ತೋರಿಸಲಾಗಿದೆ. ಈ ನಮೂನೆಗಳನ್ನು ಹೊರತುಪಡಿಸಿ ಇತರೆ ಯಾವುದೇ ನಮೂನೆಗಳಲ್ಲಿ ಸಲ್ಲಿಸಲ್ಪಡುವ ಮೀಸಲಾತಿ ಪ್ರಮಾಣ ಪತ್ರಗಳನ್ನು ತಿರಸ್ಕರಿಸಲಾಗುವುದು. ಅರ್ಜಿ ಸಲ್ಲಿಸಲು ನಿಗದಿಪಡಿಸಿದ ಕೊನೆಯ ದಿನಾಂಕದೊಳಗೆ ಪಡೆದಿಟ್ಟುಕೊಂಡಿರತಕ್ಕದ್ದು, ಮೀಸಲಾತಿ ಪ್ರಮಾಣ ಪತ್ರ ಜಾರಿ ಮಾಡಿದ ದಿನಾಂಕವನ್ನು ತಪ್ಪದೇ ಅರ್ಜಿಯ ಸಂಬಂಧಪಟ್ಟ ಅಂಕಣದಲ್ಲಿ ನಮೂದಿಸತಕ್ಕದು ಹಾಗೂ ಅದೇ ಪ್ರಮಾಣ ಪತ್ರವನ್ನು ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ಹಾಜರುಪಡಿಸತಕ್ಕದ್ದು (ಅನುಬಂಧ–1)

**5. ಗ್ರಾಮೀಣ ಅಭ್ಯರ್ಥಿ:**ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 08 ಸೇನೆನಿ 2001 ದಿ: 13–02–2001 ರನ್ವಯ ಗ್ರಾಮೀಣ ಮೀಸಲಾತಿಯನ್ನು ಕೋರುವ ಅಭ್ಯರ್ಥಿಗಳು ಪ್ರಸ್ತುತ ಚಾಲ್ತಿಯಲ್ಲಿರುವ ನಿಯಮಗಳ ರೀತ್ಯಾ 1 ರಿಂದ 10ನೇ ತರಗತಿಯವರೆಗೆ ಗ್ರಾಮೀಣ ಮೀಸಲಾತಿಗೆ ಒಳಪಡುವ ಪ್ರದೇಶಗಳಲ್ಲಿ ವ್ಯಾಸಂಗ ಮಾಡಿ ಉತ್ತೀರ್ಣರಾಗಿರುವವರು ಈ ಮೀಸಲಾತಿಯನ್ನು ಪಡೆಯಲು ಅರ್ಹರು. ಗ್ರಾಮೀಣ ಮೀಸಲಾತಿ ಪ್ರಮಾಣ ಪತ್ರಗಳಲ್ಲಿ ಕ್ಷೇತ್ರ ಶಿಕ್ಷಣಾಧಿಕಾರಿಗಳಿಂದ ಖಡ್ಡಾಯವಾಗಿ ಮೇಲು ಸಹಿ ಮಾಡಿಸಿರಬೇಕು. ಅರ್ಜಿ ಸಲ್ಲಿಸಲು ನಿಗದಿಪಡಿಸಿದ ಕೊನೆ ದಿನಾಂಕದೊಳಗೆ ಪಡೆದಿಟ್ಟುಕೊಂಡಿರತಕ್ಕದ್ದು. ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ತಪ್ಪದೇ ಹಾಜರುಪಡಿಸತಕ್ಕದ್ದು, ತಪ್ಪಿದಲ್ಲಿ ಅಂತಹ ಅಭ್ಯರ್ಥಿಗಳ ಮೀಸಲಾತಿಯನ್ನು ರದ್ದುಪಡಿಸಲಾಗುವುದು. (ಇತರೆ ನಮೂನೆಗಳಲ್ಲಿ ಸಲ್ಲಿಸಲ್ಪಡುವ ಮೀಸಲಾತಿ ಪ್ರಮಾಣ ಪತ್ರಗಳನ್ನು ತಿರಸ್ಕರಿಸಲಾಗುವುದು ಹಾಗೂ ಅಂತಹವರು ಗ್ರಾಮೀಣ ಮೀಸಲಾತಿಗೆ ಸಹ ಅನರ್ಹರಾಗುತ್ತಾರೆ. ಈ ಪ್ರಮಾಣ ಪತ್ರಗಳ ನಮೂನೆಗಳನ್ನು ಈ ಸೂಚನೆಗಳಿಗೆ ಅನಬಂಧಿಸಲಾಗಿದೆ (ಅನುಬಂಧ–2).

**6. ಅಂಗವಿಕಲ ಅಭ್ಯರ್ಥಿ:** ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್ 50 ಎಸ್‌ಆರ್‌ಆರ್ 2000 ದಿ: 03–09–2005 ರಲ್ಲಿ ರಾಜ್ಯ ಸಿವಿಲ್ ಸೇವೆಗಳ ಸಮೂಹ–'ಎ' ಮತ್ತು 'ಬಿ' ಗುಂಪಿನ ಹುದ್ದೆಗಳಿಗೆ ಶೇಡಕ 3 ರಷ್ಟು ( ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್ 21 ಎಸ್‌ಆರ್‌ಆರ್ 2008 ದಿ: 03–08–2009 ರ ಅನುಸೂಚಿಯಡಿ ಸೇರ್ಪಡೆ ಮಾಡಲಾಗಿರುವ ಇಲಾಖೆಗಳು) ಮತ್ತು ಸಮೂಹ 'ಸಿ' ಗುಂಪಿನ ಹುದ್ದೆಗಳಿಗೆ ಶೇಕಡ 5 ರಷ್ಟು (ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್ 52 ಎಸ್‌ಆರ್‌ಆರ್ 99 ದಿ: 29–11–2002ರ ಅನುಸೂಚಿಯಡಿ ಸೇರ್ಪಡಿಸಲಾಗಿರುವ ಇಲಾಖೆಗಳು) ಹುದ್ದೆಗಳನ್ನು ಅಂಗವಿಕಲರಿಗೆ ಮೀಸಲಾತಿ ಕಲ್ಪಿಸಿದ್ದು, ಇದರನ್ವಯ ಶೇಕಡ 40 ಕ್ಕಿಂತ ಕಡಿಮೆ ಇಲ್ಲದಂತಹ ಅಂಗವಿಕಲತೆಯುಳ್ಳ ಅಭ್ಯರ್ಥಿಗಳು ಮಾತ್ರ ಈ ಮೀಸಲಾತಿಯನ್ನು ಕೋರಲು ಅರ್ಹರು. ಸರ್ಕಾರದ ಅಧಿಕೃತ ಜ್ಞಾಪನ ಸಂಖ್ಯೆ: ಸಿಆಸುಇ 115 ಸೇನೆನಿ 2005 ದಿ: 19–11–2005 ರಲ್ಲಿ ನಿಗದಿಪಡಿಸಿರುವ ನಮೂನೆಯಲ್ಲಿ ಅಂಗವಿಕಲತೆ ಬಗ್ಗೆ ಜಿಲ್ಲಾ ಮಟ್ಟದ ವೈದ್ಯಕೀಯ ಮಂಡಳಿಯಿಂದ ಪ್ರಮಾಣ ಪತ್ರವನ್ನು ಅರ್ಜಿ ಸಲ್ಲಿಸಲು ನಿಗದಿಪಡಿಸಿದ ಕೊನೆಯ ದಿನಾಂಕದೊಳಗೆ ಪಡೆದಿಟ್ಟುಕೊಂಡಿರತಕ್ಕದ್ದು ಮೂಲ ದಾಖಲಾತಿಗಳನ್ನು ಪರಿಶೀಲನೆಗೆ ತಪ್ಪದೇ ಹಾಜರುಪಡಿಸತಕ್ಕದ್ದು, ತಪ್ಪದಲ್ಲಿ ಅಂತಹ ಅಭ್ಯರ್ಥಿಗಳ ಮೀಸಲಾತಿಯನ್ನು ರದ್ದುಪಡಿಸಲಾಗುವುದು. ಇತರೆ ಯಾವುದೇ ನಮೂನೆಯಲ್ಲಿ ಅಂಗವಿಕಲತೆಯ ಬಗ್ಗೆ ಪಡೆಯಲಾಗಿರುವ ಪ್ರಮಾಣ ಪತ್ರಗಳನ್ನು/ಗುರುತಿನ ಚೀಟಿಯ ಪ್ರತಿಗಳನ್ನು ಪರಿಗಣಿಸಲು ಬರುವುದಿಲ್ಲ. ಈ ಪ್ರಮಾಣ ಪತ್ರದ ನಮೂನೆಯನ್ನು ಈ ಸೂಚನೆಗಳಿಗೆ ಅನುಬಂಧಿಸಲಾಗಿದೆ (ಅನಬಂಧ–3).

(ಎ) ಅರ್ಹ ಅಭ್ಯರ್ಥಿಗಳಿಗೆ ಮೂಲ ದಾಖಲಾತಿ ಪರಿಶೀಲನೆಗೆ ಹಾಜರಾಗುವ ಪತ್ರವನ್ನು ಅಂಚೆ ಮೂಲಕ ಕಳುಹಿಸಲಾಗುವುದು. ಸದರಿ ಪತ್ರವು ಸ್ವೀಕರಿಸದೆ ಇದ್ದಲ್ಲಿ ಅಂತರ್ಜಾಲದಲ್ಲಿ ಬಿತ್ತರಿಸಲಾಗುವ ಪ್ರತಿಯನ್ನು ಡೌನ್‌ಲೋಡ್ ಮಾಡಿಕೊಂಡು ನಿಗದಿತ ದಿನಾಂಕದಂದು ಹಾಜರಾಗತಕ್ಕದ್ದು.

**7. ವ್ಯಾಸಂಗ ಪ್ರಮಾಣ ಪತ್ರದ ಬಗ್ಗೆ:** ಕರ್ನಾಟಕ ರಾಜ್ಯದಲ್ಲಿ ಹತ್ತು ವರ್ಷಗಳಿಗೆ ಕಡಿಮೆ ಇಲ್ಲದಂತೆ ಅಂದರೆ ಒಂದನೇ ತರಗತಿಯಿಂದ 10ನೇ ತರಗತಿಯವರೆಗೆ ವ್ಯಾಸಂಗ ಮಾಡದಿರುವ ಯಾವುದೇ ಅಭ್ಯರ್ಥಿಯು ಈ ನಿಯಮಗಳ ಅಡಿಯಲ್ಲಿ ಆಯ್ಕೆಗೆ ಅರ್ಹರಾಗುವುದಿಲ್ಲ. ಅಭ್ಯರ್ಥಿಗಳು 10 ವರ್ಷ ಕರ್ನಾಟಕ ರಾಜ್ಯದಲ್ಲಿ ವ್ಯಾಸಂಗ ಮಾಡಿರುವ ಬಗ್ಗೆ ಸಂಬಂಧಪಟ್ಟ ಶಾಲೆಗಳ ಮುಖ್ಯೋಪಾಧ್ಯಾಯರಿಂದ ಪ್ರಮಾಣ ಪತ್ರಗಳನ್ನು ಪಡೆದು ಅರ್ಜಿಗಳನ್ನು ಸಲ್ಲಿಸಲು ನಿಗದಿಪಡಿಸಲಾಗಿರುವ ಕೊನೆಯ ದಿನಾಂಕದೊಳಗೆ ಪಡೆದಿಟ್ಟುಕೊಂಡಿರತಕ್ಕದ್ದು.

**8. ಸರ್ಕಾರಿ ಸೇವೆಯಲ್ಲಿರುವ ನೌಕರರಿಗೆ:** ಅಭ್ಯರ್ಥಿಯು ಕರ್ನಾಟಕ ರಾಜ್ಯ ಸರ್ಕಾರದಲ್ಲಿ ಅಥವಾ ಸ್ಥಳೀಯ ಪ್ರಾಧಿಕಾರದಲ್ಲಿ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಯಾದ ಅಥವಾ ರಾಜ್ಯ ಅಧಿನಿಯಮದ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಗೊಂಡು ಕರ್ನಾಟಕ ರಾಜ್ಯ ಸರ್ಕಾರದ ಸ್ವಾಮ್ಯ ಅಥವಾ ನಿಯಂತ್ರಣದಲ್ಲಿರುವ ನಿಗಮದಲ್ಲಿ ಹುದ್ದೆ ಹೊಂದಿರುವ ನೌಕರರು(ಪ್ರಮಾಣ ಪತ್ರವನ್ನು ಸಂಬಂಧಪಟ್ಟ ಇಲಾಖೆಯಿಂದ ಪಡೆದಿಟ್ಟುಕೊಂಡಿರತಕ್ಕದ್ದು) ಅನುಬಂದ–4.

**9. ವಿಶೇಷ ಸೂಚನೆಗಳು:**

1) ಹುದ್ದೆಗೆ ನಿಗದಿಪಡಿಸಿದ ಶುಲ್ಕ (ಅರ್ಜಿಯನ್ನು ಭರ್ತಿ ಮಾಡಿದ ನಂತರ ಪಾವತಿಸತಕ್ಕದ್ದು) ಪಾವತಿ ರಸೀತಿ.

2) ಹುದ್ದೆಗಳಿಗೆ ನಿಗದಿಪಡಿಸಲಾದ ವಿದ್ಯಾರ್ಹತೆಯ ಎಲ್ಲಾ ವರ್ಷಗಳ ಅಂಕಪಟ್ಟಿಗಳು

3) ಜನ್ಮ ದಿನಾಂಕವನ್ನು ನಮೂದಿಸಿರುವ ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯ ಪ್ರಮಾಣ ಪತ್ರ / ವರ್ಗಾವಣೆ ಪ್ರಮಾಣ ಪತ್ರ ಜನನ ದಿನಾಂಕವನ್ನು ತೋರಿಸುವ ಸಂಚಿತ ದಾಖಲೆಯ ಉದ್ಧೃತ ಭಾಗ

4) ನಿರಾಪೇಕ್ಷಣಾ ಪತ್ರ (No Objection Certificate) (ಸರ್ಕಾರಿ ಸೇವೆಯಲ್ಲಿರುವ ಅಭ್ಯರ್ಥಿಗಳಿಗೆ)

5) ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ, ಪ್ರಸ್ತುತ ಚಾಲ್ತಿಯಲ್ಲಿರುವ ನಮೂನೆಗಳಲ್ಲಿ,

6) ಗ್ರಾಮೀಣ ಮೀಸಲಾತಿ ಪ್ರಮಾಣ ಪತ್ರ ನಮೂನೆ–1 ಮತ್ತು 2 ರಲ್ಲಿ (ಮೀಸಲಾತಿ ಕೋರಿದ್ದಲ್ಲಿ)

7) ಅಂಗವಿಕಲ ಮೀಸಲಾತಿ ಪ್ರಮಾಣ ಪತ್ರ (ವಯೋಮಿತಿ ಸಡಿಲಿಕೆಗಾಗಿ ಮೀಸಲಾತಿ ಕೋರಿದ್ದಲ್ಲಿ)

**10. ದುರ್ನಡತೆ:** ಒಬ್ಬ ಅಭ್ಯರ್ಥಿಯು ನಕಲಿ ವ್ಯಕ್ತಿಯಾಗುರುವನೆಂದು ಅಥವಾ ಖೋಟಾ ದಸ್ತಾವೇಜು ಅಥವಾ ತಿದ್ದಲಾದ ದಸ್ತಾವೇಜುಗಳನ್ನು ಸಲ್ಲಿಸಿರುವನೆಂದುಅಥವಾ ತಪ್ಪು ಅಥವಾ ಸುಳ್ಳು ಹೇಳಿಕೆ ನೀಡಿರುವನೆಂದು ಅಥವಾ ವಾಸ್ತವಿಕ ಮಾಹಿತಿಯನ್ನು ಮರೆಮಾಚಿರುವನೆಂದು ಅಥವಾ ನೇಮಕಾತಿ ಉದ್ದೇಶಗಳಿಗಾಗಿ ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ಅನುಚಿತ ಮಾರ್ಗವನ್ನು ಅನುಸರಿಸುತ್ತಿರುವನೆಂದು ಅಥವಾ ಅನುಸರಿಸಲು ಪ್ರಯತ್ನಿಸಿರುವನೆಂದು ಅಥವಾ ಅವರ ನೇಮಕಾತಿಯ ಸಂಬಂಧದಲ್ಲಿ ಯಾವುದೇ ಇತರೆ ಅಕ್ರಮ ಮತ್ತು ಅನುಚಿತ ಮಾರ್ಗ ಅವಲಂಬಿಸಿರುವನೆಂದು, ಕಂಡುಬಂದಲ್ಲಿ ಅವನು / ಅವಳು ಸ್ವತ: ಕ್ರಿಮಿನಲ್ ವ್ಯವಹರಣೆಗಳಿಗೆ ಮತ್ತು ಶಿಸ್ತು ಕ್ರಮಕ್ಕೆ ಒಳಪಡುವುದಲ್ಲದೆ; ಹುದ್ದೆಯ ಮೂಲ ದಾಖಲಾತಿ ಪರಿಶೀಲನಾ/ಆಯ್ಕೆಯಿಂದ ಅಭ್ಯರ್ಥಿತ್ವವನ್ನು ರದ್ದುಪಡಿಸಲಾಗುವುದು.

**ಸದಸ್ಯ ಕಾರ್ಯದರ್ಶಿ ನೇಮಕಾತಿ ಸಮಿತಿ**
**ಹಾಗೂ ಮುಖ್ಯ ಆಡಳಿತಾಧಿಕಾರಿಗಳು,**
**ಆಯುಷ್ ಇಲಾಖೆ.**

ಆಯುಷ್ ಇಲಾಖೆ ಆಯುಷ್ ನಿರ್ದೇಶನಾಲಯ, ಧನ್ವಂತರಿ ರಸ್ತೆ, ಬೆಂಗಳೂರು– 560 009.

ಅಧಿಸೂಚನೆ ಸಂಖ್ಯೆ:ಆಯುಷ್/170/ಸಿಬ್ಬಂದಿ(2)/2013–14

**Name of the Post: Staff Nurse in the Department of Ayush -05 posts**

ಆಯುಷ್ ಇಲಾಖೆಯಲ್ಲಿ ಶುಶ್ರೂಷಕಿಯರ – 5 ಹುದ್ದೆಗಳು.

ಪರಿಶಿಷ್ಠ ಪಂಗಡ ಅಭ್ಯರ್ಥಿಗಳು ಮಾತ್ರ ಅರ್ಜಿ ಸಲ್ಲಿಸಬೇಕು

**Personal details**

Full Name of the Candidate (As in SSLC or 10 Std Marks Card)
ಅಭ್ಯರ್ಥಿಯ ಪೂರ್ಣ ಹೆಸರು (ಎಸ್.ಎಸ್.ಎಲ್.ಸಿ.ಅಥವಾ 10ನೇ ತರಗತಿ ಅಂಕಪಟ್ಟಿಯಲ್ಲಿರುವಂತೆ)

Father's Name:
ತಂದೆಯ ಹೆಸರು:

Mother's Name:
ತಾಯಿಯ ಹೆಸರು:

Spouse's Name (if married):
ಗಂಡ/ಹೆಂಡತಿಯ ಹೆಸರು (ವಿವಾಹವಾಗಿದ್ದರೆ)

Date of Birth: YYY MM DD
ಹುಟ್ಟಿದ ದಿನಾಂಕ:

Gender
ಲಿಂಗ:

## Contact Details

Postal Address:

Native District:
Pin Code:
ಪಿನ್ ಸಂಖ್ಯೆ:

Email (Optional):
ಇ–ಮೇಲ್:

## Qualification Details

Must have passed in SSLC or equivalent Qualification with Diploma in Nursing 3 ½ years course of an institution recognized by the Govt. of Karnataka.

Date of Passing/Date of issue of Certificate: YYY MM DD

Class secured

Name of the board/institute/university:

Maximum Marks/SGPA in all years /Semesters:

Total marks secured/SGPA in all years/Semesters:

Aggregate Percentage (%) secured:

Do you possess a 3 ½ years Diploma in Nursing?
Name of the board/institute/university:

Date of pass: YYY MM DD

Class secured:

Maximum marks/SGPA in all years/semesters:

Total marks/SGPA secured in all years/Semesters:

Aggregate Percentage (%) secured:

Date of Registration in Nursing Council: YYY MM DD

## CategoryDetails

Reservation claimed :

**Rural Candidate Details:**

Rural Candidate: Yes No.
ಗ್ರಾಮೀಣ ಅಭ್ಯರ್ಥಿಯೇ:

Note: ಗ್ರಾಮೀಣ ಅಭ್ಯರ್ಥಿ ಎಂದರೆ ನಿಯಮಗಳ ರೀತ್ಯಾ ಗ್ರಾಮೀಣ ಮೀಸಲಾತಿಗೆ ಒಳಪಡುವ ಪ್ರದೇಶಗಳಲ್ಲಿ 01ನೇ ತರಗತಿಯಿಂದ 10ನೇ ತರಗತಿಯವರೆಗೆ ವ್ಯಾಸಂಗ ಮಾಡಿ ಉತ್ತೀರ್ಣರಾಗಿ ರುವವರು ನಮೂನೆ–02ರಲ್ಲಿ ಮತ್ತು ಸಾಮಾನ್ಯ ಅರ್ಹತೆ ಅಭ್ಯರ್ಥಿಗಳು ನಮೂನೆ–01 ಮತ್ತು 02 ರಲ್ಲಿ ಸಂಬಂಧಪಟ್ಟ ಪ್ರಾಧಿಕಾರದಿಂದ ಅರ್ಜಿ ಸಲ್ಲಿಸುವ ಕೊನೆಯ ದಿನಾಂಕದೊಳಗೆ ಚಾಲ್ತಿಯಲ್ಲಿರುವಂತೆ ಪ್ರಮಾಣ ಪತ್ರ ಪಡೆದಿರಬೇಕು.

Physically Handicapped/Disabled Candidate Details

Physically Handicapped/Disabled (PH/D): Yes No.

ಅಂಗವಿಕಲ ಅಭ್ಯರ್ಥಿಯೇ:

Government Employee Details

Government Employee
ಸರ್ಕಾರಿ ನೌಕರರೇ: Yes No.

Are You Claiming for age relaxation: ವಯೋಮಿತಿ ಸಡಿಲಿಕೆ ಕೋರುವಿರಾ:

Age relaxation : Yes No.
ವಯೋಮಿತಿ ಸಡಿಲಿಕೆ:

Relaxation Type:

## Declaration:

I hereby declare that all contents entered in this application are true, complete and correct to the best of my knowledge and belief. I have read the rules and understand that in the event of any information being found false or ineligibility being detected before or after the selection, my application is liable to be rejected. Action can be taken against me by the Government under rule 20 of the Karnataka Civil Services (General Recruitment) Rules1977 as amended from time to time. I have read the rules and instructions carefully and hereby undertake to abide by them. I further declare that I fulfill all the eligibility conditions regarding age, educational qualification, reservation etc., wherever applicable, prescribed for the post.

**Signature**

**ಆಯುಷ್ ಇಲಾಖೆ ಆಯುಷ್ ನಿರ್ದೇಶನಾಲಯ,ಧನ್ವಂತರಿ ರಸ್ತೆ, ಬೆಂಗಳೂರು– 560 009.**

**ಅಧಿಸೂಚನೆ ಸಂಖ್ಯೆ:ಆಯುಷ್/170/ಸಿಬ್ಬಂದಿ(2)/2013–14**

**Name of the Post: pharmacist in the Department of Ayush -05 posts**

**ಆಯುಷ್ ಇಲಾಖೆಯಲ್ಲಿ ಔಷಧ ವಿತರಕರು – 09 ಹುದ್ದೆಗಳು.**

**ಪರಿಶಿಷ್ಟ ಜಾತಿ ಅಭ್ಯರ್ಥಿಗಳು ಮಾತ್ರ ಅರ್ಜಿ ಸಲ್ಲಿಸಬೇಕು**

## Personal details

Full Name of the Candidate (As in SSLC or 10 Std Marks Card)
ಅಭ್ಯರ್ಥಿಯ ಪೂರ್ಣ ಹೆಸರು (ಎಸ್.ಎಸ್.ಎಲ್.ಸಿ.ಅಥವಾ 10ನೇ ತರಗತಿ ಅಂಕಪಟ್ಟಿಯಲ್ಲಿರುವಂತೆ)

Father's Name:
ತಂದೆಯ ಹೆಸರು:

Mother's Name:
ತಾಯಿಯ ಹೆಸರು:

Spouse's Name (if married):
ಗಂಡ/ಹೆಂಡತಿಯ ಹೆಸರು (ವಿವಾಹವಾಗಿದ್ದರೆ)

Date of Birth: YYY MM DD
ಹುಟ್ಟಿದ ದಿನಾಂಕ:

Gender
ಲಿಂಗ:

## Contact Details

Postal Address:

Native District:

Pin Code:
ಪಿನ್ ಸಂಖ್ಯೆ:

Email (Optional):
ಇ–ಮೇಲ್:

## Qualification Details

Must be holder of Diploma in Pharmacy (AYUSH) from a recognized institution.

Provided that if no candidates is available then a candidate who passed PUC with Science subject or equivalent qualification and Diploma in Pharmacy from institution recognized by Government of Karnataka.

Date of Passing/Date of issue of Certificate: YYY MM DD

Class secured

Name of the board/institute/university:

Maximum Marks/SGPA in all years /Semesters:

Total marks secured/SGPA in all years/Semesters:

Aggregate Percentage (%) secured:

Do you possess a Diploma in Pharmacy?

Name of the board/institute/university:

Date of pass: YYY MM DD

Class secured:

Maximum marks/SGPA in all years/semesters:

Total marks/SGPA secured in all years/Semesters:

Aggregate Percentage (%) secured:

Date of Registration in Nursing Council: YYY MM DD

## CategoryDetails

Reservation claimed :

## Rural Candidate Details:

Rural Candidate: Yes No.
ಗ್ರಾಮೀಣ ಅಭ್ಯರ್ಥಿಯೇ:

**Note:** ಗ್ರಾಮೀಣ ಅಭ್ಯರ್ಥಿ ಎಂದರೆ ನಿಯಮಗಳ ರೀತ್ಯಾ ಗ್ರಾಮೀಣ ಮೀಸಲಾತಿಗೆ ಒಳಪಡುವ ಪ್ರದೇಶಗಳಲ್ಲಿ 01ನೇ ತರಗತಿಯಿಂದ 10ನೇ ತರಗತಿಯವರೆಗೆ ವ್ಯಾಸಂಗ ಮಾಡಿ ಉತ್ತೀರ್ಣರಾಗಿ ರುವವರು ನಮೂನೆ-02ರಲ್ಲಿ ಮತ್ತು ಸಾಮಾನ್ಯ ಅರ್ಹತೆ ಅಭ್ಯರ್ಥಿಗಳು ನಮೂನೆ-01 ಮತ್ತು 02 ರಲ್ಲಿ ಸಂಬಂಧಪಟ್ಟ ಪ್ರಾಧಿಕಾರದಿಂದ ಅರ್ಜಿ ಸಲ್ಲಿಸುವ ಕೊನೆಯ ದಿನಾಂಕದೊಳಗೆ ಚಾಲ್ತಿಯಲ್ಲಿರುವಂತೆ ಪ್ರಮಾಣ ಪತ್ರ ಪಡೆದಿರಬೇಕು.

Physically Handicapped/Disabled Candidate Details

Physically Handicapped/Disabled (PH/D): Yes No.
ಅಂಗವಿಕಲ ಅಭ್ಯರ್ಥಿಯೇ:

Government Employee Details

Government Employee
ಸರ್ಕಾರಿ ನೌಕರರೇ: Yes No.

Are You Claiming for age relaxation: ವಯೋಮಿತಿ ಸಡಿಲಿಕೆ ಕೋರುವಿರಾ:

Age relaxation : Yes No.
ವಯೋಮಿತಿ ಸಡಿಲಿಕೆ:

Relaxation Type:

## Declaration:

I hereby declare that all contents entered in this application are true, complete and correct to the best of my knowledge and belief. I have read the rules and understand that in the event of any information being found false or ineligibility being detected before or after the selection, my application is liable to be rejected. Action can be taken against me by the Government under rule 20 of the Karnataka Civil Services (General Recruitment) Rules1977 as amended from time to time. I have read the rules and instructions carefully and hereby undertake to abide by them. I further declare that I fulfill all the eligibility conditions regarding age, educational qualification, reservation etc., wherever applicable, prescribed for the post.

**PR.94** **Signature.**
**SC.10**